# ಕರ್ನಾಟಕ ರಾಜ್ಯಪತ್ರ

ಅಧಿಕೃತವಾಗಿ ಪ್ರಕಟಿಸಲಾದುದು

| ಸಂಪುಟ ೧೪೭ | ಬೆಂಗಳೂರು, ಗುರುವಾರ, ಡಿಸೆಂಬರ್ ೨೭, ೨೦೧೨ (ಪುಷ್ಯ ೬, ಶಕ ವರ್ಷ ೧೯೩೪) | ಸಂಚಿಕೆ ೫೧ |
|---|---|---|


## ಭಾಗ – ೪ಎ

## ರಾಜ್ಯದ ವಿಧೇಯಕಗಳ ಮತ್ತು ಅವುಗಳ ಮೇಲೆ ಪರಿಶೀಲನಾ ಸಮಿತಿಯ ವರದಿಗಳು, ರಾಜ್ಯದ ಅಧಿನಿಯಮಗಳು ಮತ್ತು ಅಧ್ಯಾದೇಶಗಳು, ಕೇಂದ್ರದ ಮತ್ತು ರಾಜ್ಯದ ಶಾಸನಗಳ ಮೇರೆಗೆ ರಾಜ್ಯ ಸರ್ಕಾರವು ಹೊರಡಿಸಿದ ಸಾಮಾನ್ಯ ಶಾಸನಬದ್ಧ ನಿಯಮಗಳು ಮತ್ತು ರಾಜ್ಯಾಂಗದ ಮೇರೆಗೆ ರಾಜ್ಯಪಾಲರು ಮಾಡಿದ ನಿಯಮಗಳು, ಹಾಗೂ ಕರ್ನಾಟಕ ಉಚ್ಚ ನ್ಯಾಯಾಲಯವು ಮಾಡಿದ ನಿಯಮಗಳು

**ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಸಚಿವಾಲಯ**

**ಅಧಿಸೂಚನೆ**

**ಸಂಖ್ಯೆ: ಸಿಆಸುಇ 15 ಸೇಇವಿ 2011 ಬೆಂಗಳೂರು, ದಿನಾಂಕ: 03–09–2012.**

ಕರ್ನಾಟಕ ನಾಗರೀಕ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಮಗಳು, 1957 ಇದನ್ನು ಮತ್ತಷ್ಟು ತಿದ್ದುಪಡಿ ಮಾಡುವುದಕ್ಕೆ ದಿನಾಂಕ: 30–06–2012ರ ಅಧಿಸೂಚನೆ ಸಂಖ್ಯೆ: ಸಿಆಸುಇ 15 ಸೇಇವಿ 2011ರಲ್ಲಿ ಪ್ರಕಟಿಸಿರುವ ಈ ಮುಂದಿನ ನಿಯಮಗಳ ಕರಡನ್ನು ಅಧಿಕೃತ ರಾಜ್ಯಪತ್ರದಲ್ಲಿ ಇದರ ಪ್ರಕಟಣೆಯ ದಿನಾಂಕದಿಂದ 15 ದಿನಗಳೊಳಗಾಗಿ ಅದರಿಂದ ಬಾಧಿತರಾಗುವ ಸಂಭವವಿರುವ ಎಲ್ಲ ವ್ಯಕ್ತಿಗಳಿಂದ ಆಕ್ಷೇಪಣೆಗಳನ್ನು ಮತ್ತು ಸಲಹೆಗಳನ್ನು ಆಹ್ವಾನಿಸಿ ದಿನಾಂಕ: 30–06–2012ರ ಕರ್ನಾಟಕ ರಾಜ್ಯಪತ್ರದ ಭಾಗ–ivಎ (ಸಂ.445)ರಲ್ಲಿ ಕರ್ನಾಟಕ ರಾಜ್ಯ ನಾಗರೀಕ ಸೇವೆಗಳ ಅಧಿನಿಯಮ, 1978 (1990ರ ಕರ್ನಾಟಕ ಅಧಿನಿಯಮ 14)ರ 3ನೇ ಪ್ರಕರಣದ (2)ನೇ ಉಪ ಪ್ರಕರಣದ (ಎ) ಖಂಡದ ಮೂಲಕ ಅಗತ್ಯಪಡಿಸಲಾದಂತೆ ಪ್ರಕಟಿಸಲಾಗಿರುವುದರಿಂದ;

ಸದರಿ ರಾಜ್ಯ ಪತ್ರವನ್ನು 30–06–2012 ರಂದು ಸಾರ್ವಜನಿಕರಿಗೆ ಲಭ್ಯವಾಗುವಂತೆ ಮಾಡಿರುವುದರಿಂದ;

ಮತ್ತು, ಸದರಿ ಕರಡಿನ ಬಗ್ಗೆ ಯಾವುದೇ ಆಕ್ಷೇಪಣೆ/ ಸಲಹೆಗಳು ಸ್ವೀಕೃತವಾಗದಿರುವುದರಿಂದ;

ಈಗ ಕರ್ನಾಟಕ ರಾಜ್ಯ ನಾಗರೀಕ ಸೇವೆಗಳ ಅಧಿನಿಯಮ, 1978 (1990ರ ಕರ್ನಾಟಕ ಅಧಿನಿಯಮ 14)ರ 8ನೇ ಪ್ರಕರಣದೊಂದಿಗೆ ಓದಿಕೊಂಡ 3ನೇ ಪ್ರಕರಣದ (1)ನೇ ಉಪ ಪ್ರಕರಣದ ಮೂಲಕ ಪ್ರದತ್ತವಾದ ಅಧಿಕಾರಗಳನ್ನು ಚಲಾಯಿಸಿ, ಕರ್ನಾಟಕ ಸರ್ಕಾರವು ಈ ಮೂಲಕ ಈ ಕೆಳಕಂಡ ನಿಯಮಗಳನ್ನು ರಚಿಸುತ್ತದೆ ಎಂದರೆ:–

**ನಿಯಮಗಳು**

1. **ಹೆಸರು ಮತ್ತು ಪ್ರಾರಂಭ:–** (1) ಈ ನಿಯಮಗಳನ್ನು ಕರ್ನಾಟಕ ನಾಗರೀಕ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) (ತಿದ್ದುಪಡಿ) ನಿಯಮಗಳು, 2012 ಎಂದು ಕರೆಯತಕ್ಕದ್ದು.

   (2) ಈ ನಿಯಮವು ಅಧಿಕೃತ ರಾಜ್ಯಪತ್ರದಲ್ಲಿ ಪ್ರಕಟವಾದ ದಿನಾಂಕದಿಂದ ಜಾರಿಗೆ ಬರತಕ್ಕದ್ದು.

2. **ನಿಯಮ 15 ಕ್ಕೆ ತಿದ್ದುಪಡಿ:–** ಕರ್ನಾಟಕ ನಾಗರೀಕ ಸೇವಾ (ವರ್ಗಿಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಮಗಳು, 1957ರ ನಿಯಮ 15ರ

(i) ಉಪನಿಯಮ (2ಬಿ) ಖಂಡ (i)ರ ನಂತರ ಕೆಳಕಂಡ ಪರಂತುಕವನ್ನು ಪ್ರತಿಸ್ಥಾಪಿಸತಕ್ಕದ್ದು, ಅಂದರೆ:–

"ಪರಂತು, ಆಯುಕ್ತರು, ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ಇವರು ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ನಿಯೋಜನೆಯ ಮೇಲೆ ಕರ್ತವ್ಯ ನಿರ್ವಹಿಸುತ್ತಿರುವ ಗುಂಪು 'ಬಿ' ಗುಂಪು 'ಸಿ' ಅಥವಾ ಗುಂಪು 'ಡಿ' ವೃಂದದ ನೌಕರರ ಪ್ರಕರಣಗಳಿಗೆ ಸಂಬಂಧಿಸಿದಂತೆ ಇನ್ನು ಮುಂದೆ ನೇಮಕಾತಿ ಪ್ರಾಧಿಕಾರದ ಕರ್ತವ್ಯಗಳನ್ನು ನಿರ್ವಹಿಸತಕ್ಕದ್ದು"

(ii) ಉಪನಿಯಮ (3)ರ ಪರಂತುಕದಡಿ ಇರುವ ಉಪ ಖಂಡ (i) ರಲ್ಲಿ "ಉಪನಿಯಮ (2ಎ) ರ ಖಂಡ (ii)ರ ಉಪಖಂಡ (ಎ) ಅಥವಾ" ಎಂಬ ಪದಗಳ ನಂತರ "ಖಂಡ (i)ರಡಿಯಿರುವ ಪರಂತುಕ ಮತ್ತು" ಎಂಬ ಪದಗಳನ್ನು ಪ್ರತಿಸ್ಥಾಪಿಸತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಡಾ: ಮಂಗಳ. ಜಿ. ಎಸ್.**

ಸರ್ಕಾರದ ಅಧೀನ ಕಾರ್ಯದರ್ಶಿ,

ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ, (ಸೇವಾ ನಿಯಮಗಳು–1)

## PERSONNEL AND ADMINISTRATIVE REFORMS SECRETARIAT

### NOTIFICATION

### NO: DPAR 15 SDE 2011 BANGALORE, DATED: 03-09- 2012

Whereas the draft of the following rules further to amend the Karnataka Civil Services (Classification, Control and Appeal) Rules, 1957 was published as required by clause (a), sub-section (2) of Section 3 of the Karnataka State Civil Services Act, 1978 (Karnataka Act 14 of 1990) in Notification No. DPAR 15 SDE 2011, Dated: 30-6-2012, in part IVA (P.R. No. 445) of the Karnataka Gazette dated: 30-06-2012 inviting objections and suggestions from all persons likely to be affected thereby within fifteen days from the date of its publication in the Official Gazette.

Whereas, the said Gazette, was made available to the public on 30-6-2012.

And Whereas, no objections, and suggestions have been received in this behalf by the State Government.

Now, therefore, in exercise of the powers conferred by sub-section (1) of section 3 read with section 8 of the Karnataka State Civil Services Act, 1978 (Karnataka Act 14 of 1990) the Government of Karnataka hereby makes the following rules, namely:-

**RULES**

**1. Short title and Commencement:- (1)** These rules may be called the Karnataka Civil Services (Classification, Control and Appeal) (Amendment) Rules, 2012.

(2) They shall come into force from the date of their publication in the official Gazette.

**2. Amendment of Rule 15**:- In the Karnataka Civil Services (Classification, Control and Appeal) Rules, 1957 in rule 15,

(i) in sub-rule (2B), after clause (i) the following proviso shall be inserted, namely:-

"provided that the Commissioner, Bruhat Bangalore Mahanagara Palike in respect of a Government Servant holding a Group 'B' Group 'C' or Group 'D' post whose services are lent to the Bruhat Bangalore Mahanagara Palike shall perform the functions of the appointing authority"

(ii) in sub-rule (3) in the proviso in clause (i) after the words "sub-clause (a) of clause (ii) of sub-rule (2A) or" the words "in the proviso to clause (i) and" shall be inserted.

By order and in the name of the Governor of Karnataka

**Dr. Mangala. G.S.**

Under Secretary to Government

DPAR (Service Rules-1)

**PR. 669**

## COMMERCE AND INDUSTRIES SECRETARIAT

### NOTIFICATION

### NO. CI 142 MMN 2011, BANGALORE, DATED: 20-11-2012

The draft of the following rules further to amend the Karnataka minor Mineral Concession Rules, 1994. Which the Government of Karnataka proposes to make in Mines and Minerals (Regulation and Development) Act, 1957 (Central Act 67 of 1957), is hereby published for the information of all persons likely to be affected thereby and notice is hereby given that the said draft will be taken in to consideration after expiry of fifteen days from the date of its publication in the official gazette.

Any objection or suggestion which may be received by the State Government from any person with respect to the said draft before the expiry of the period specified above will be considered by the State Government objections or suggestions may be addressed to the Secretary to Government, Commerce and Industries Department, Vikasa Soudha, Bangalore-560 00.

**DRAFT RULES**

**1. Title and Commencement:-** (1) These rules may be called the Karnataka Minor Mineral Concession (Amendment) Rules, 2012.

**(2) They shall come into force From the date of their publication in the official Gazette**.

**2. Amendment of Rule 31R:-** In the Karnataka Minor Mineral Concession Rules, 1994 in rule 31R, after sub rule (14), the following shall be inserted, namely:-

"Provided that the sand could be transported to Lakshadeep till 31.03.2013 under valid permits from the competent authority"

By Order and in the name of the Governor of Karnataka,

**K. VENKATESH**

Desk Officer (Mines)

Commerce and Industries Department

**PR.716**

## URBAN DEVELOPMENT SECRETARIAT

### NOTIFICATION

### NO. UDD 213 BMR 2011 (P) BANGALORE, DATED: 18-07-2012

The draft of the following Regulations further to amend the Zonal Regulations of master plan of the local planning area of BIAAPA, which the Government of Karnataka proposes to make in exercise of the powers conferred by section 13-E of the Karnataka Town and Country Planning Act 1961, is hereby published as required by the said section, for the information of all persons likely to be affected thereby and notice is hereby given that the said draft will be taken into consideration after thirty days from the date of its publication in the official Gazette.

Any objection or suggestion which may be received by the State Government from any person with respect to the said draft before the expiry of the period specified above will be considered by the State Government. Objections and Suggestions may be addressed to the Principal Secretary to Government, Urban Development Department, Vikasa Soudha, Bangalore-560001.

**DRAFT REGULATIONS**

**1. Title and Commencement.-(**1) These regulations may be called the Zonal Regulations of master plan of local planning area of BIAAPA (Amendment) Regulations, 2012.

**(**2) They shall come into force from the date of their publication in the official Gazette.

**2. Amendment of Regulation 9.3.-** In the Zonal regulations of Master plan of the local planning area of BIAAPA, in regulation 9.3, in table-2 for the words, letters and figures "The height of the buildings in BIAAPA is limited to the maximum of G+7 floor or 25 meters which ever is lower" the words the height of the buildings in BIAAPA is limited to the height permitted by Airport Authority of India, under the provisions of the Aircraft Act, 1934 (Central Act 22 of 1934) subject to maximum floor area ratio permitted by the State Government in the Zonal regulations" shall be substituted.

By Order and in the name of the Governor of Karnataka,

**S. CHANDRAPPA**

Under Secretary to Government

Urban Development Department .

**PR.715**

## ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಸಚಿವಾಲಯ

**ಕರ್ನಾಟಕ ಮಾಹಿತಿ ಹಕ್ಕು ಅಧಿನಿಯಮ, 2005 ನಿಯಮ 4(1)(ಬಿ)**

**(ಆಗಸ್ಟ್ 2012ರ ಅಂತ್ಯಕ್ಕೆ ಪರಿಷ್ಕೃತ)**

**ಸಂಖ್ಯೆ: ಲಾ 18 ಎಲ್ಎಎಂ 2012 ಬೆಂಗಳೂರು, ದಿನಾಂಕ: 12-09-2012**

**ಅಧಿಸೂಚನೆ**

ಮಾಹಿತಿ ಹಕ್ಕು ಅಧಿನಿಯಮ 2005ರ ಪ್ರಕರಣ 4(1)(ಬಿ) ಮೇರೆಗೆ ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯ ಸಚಿವಾಲಯಕ್ಕೆ ಸಂಬಂಧಿಸಿದ ಮಾಹಿತಿಯನ್ನು ಆಗಸ್ಟ್ 2012ರ ಅಂತ್ಯಕ್ಕೆ ಪರಿಷ್ಕರಿಸಿ ಅನುಬಂಧ 1ರಲ್ಲಿ ಪ್ರಕಟಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆದೇಶದ ಮೇರೆಗೆ ಮತ್ತು ಅವರ ಹೆಸರಿನಲ್ಲಿ,

**ಕೆ.ಎನ್.ಫಣೀಂದ್ರ**

ಸರ್ಕಾರದ ಪ್ರಧಾನ ಕಾರ್ಯದರ್ಶಿ,

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆ

**ಅನುಬಂಧ - 1**

**ವಿಷಯ ಸೂಚಿ**

| ಕ್ರಮ ಸಂಖ್ಯೆ | ಶಾಖೆ |
|---|---|
| 1 | ಪ್ರಧಾನ ಕಾರ್ಯದರ್ಶಿಯವರ ಆಪ್ತ ಶಾಖೆ |
| 2 | ವಿಶೇಷ ಕಾರ್ಯದರ್ಶಿಯವರ ಆಪ್ತ ಶಾಖೆ |
| 3 | ಅಪರ ಕಾನೂನು ಕಾರ್ಯದರ್ಶಿ (ಅಭಿಪ್ರಾಯ) ರವರ ಆಪ್ತ ಶಾಖೆ |
| 4 | ಅಪರ ಕಾನೂನು ಕಾರ್ಯದರ್ಶಿ-1 ರವರ ಆಪ್ತ ಶಾಖೆ |
| 5 | ಅಪರ ಕಾನೂನು ಕಾರ್ಯದರ್ಶಿ-2 ರವರ ಆಪ್ತ ಶಾಖೆ |
| 6 | ಅಪರ ಕಾನೂನು ಕಾರ್ಯದರ್ಶಿ-3 ರವರ ಆಪ್ತ ಶಾಖೆ |
| 7 | ಉಪ ಕಾರ್ಯದರ್ಶಿ (ಆಡಳಿತ-1) ರವರ ಆಪ್ತ ಶಾಖೆ |
| 8 | ಉಪ ಕಾರ್ಯದರ್ಶಿ (ಆಡಳಿತ-2) ರವರ ಆಪ್ತ ಶಾಖೆ |
| 9 | ಉಪ ಕಾರ್ಯದರ್ಶಿ (ಅಂರಾಜವಿ) ರವರ ಆಪ್ತ ಶಾಖೆ |
| 10 | ಉಪ ಕಾರ್ಯದರ್ಶಿ (ಅಭಿಪ್ರಾಯ-1) ರವರ ಆಪ್ತ ಶಾಖೆ |
| 11 | ಉಪ ಕಾರ್ಯದರ್ಶಿ (ಅಭಿಪ್ರಾಯ-2)ರವರ ಆಪ್ತ ಶಾಖೆ |
| 12 | ಉಪ ಕಾರ್ಯದರ್ಶಿ (ಅಭಿಪ್ರಾಯ-3)ರವರ ಆಪ್ತ ಶಾಖೆ |
| 13 | ವಾದೇಕ್ಷಕರು ಹಾಗೂ ಪದನಿಮಿತ್ತ ಸರ್ಕಾರದ ಉಪ ಕಾರ್ಯದರ್ಶಿರವರ ಆಪ್ತ ಶಾಖೆ |
| 14 | ಅಧೀನ ಕಾರ್ಯದರ್ಶಿ (ಆಡಳಿತ-1) ಶಾಖೆ |
| 15 | ಅಧೀನ ಕಾರ್ಯದರ್ಶಿ (ಆಡಳಿತ-2) ಶಾಖೆ |
| 16 | ಅಧೀನ ಕಾರ್ಯದರ್ಶಿ (ಮಾನವ ಹಕ್ಕುಗಳು ಶಾಖೆ) |
| 17 | ಸಹಾಯಕ ವಾದೇಕ್ಷಕರು ಹಾಗೂ ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ (ವ್ಯಾಜ್ಯ-6) ಶಾಖೆ |
| 18 | ಸಹಾಯಕ ವಾದೇಕ್ಷಕರು ಹಾಗೂ ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ (ವ್ಯಾಜ್ಯ-7) ಶಾಖೆ |

| ಕ್ರ.ಮ ಸಂಖ್ಯೆ | ಶಾಖೆ |
|---|---|
| 19 | ಶಾಖಾಧಿಕಾರಿ (ಅಂತರರಾಜ್ಯ ಜಲವಿವಾದ) ಶಾಖೆ |
| 20 | ಶಾಖಾಧಿಕಾರಿ (ಅಭಿಪ್ರಾಯ) ಶಾಖೆ |
| 21 | ಶಾಖಾಧಿಕಾರಿ (ಸ್ವೀಕೃತಿ ಮತ್ತು ರವಾನೆ) ಶಾಖೆ |

**ಕರ್ನಾಟಕ ಸರ್ಕಾರದ ಸಚಿವಾಲಯ**

**ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆ**






ಶ್ರೀಮತಿ ಎಂ. ಶ್ರೀದೇವಿ,
ಅಪರ ಕಾರ್ಯದರ್ಶಿ (ಅಭಿಪ್ರಾಯ)

ಶ್ರೀ ಮೊಹಮ್ಮದ್ ಇಸ್ಮಾಯಿಲ್, ಉಪ ಕಾರ್ಯದರ್ಶಿ (ಅಭಿಪ್ರಾಯ–1)

ಶ್ರೀ ಜಿ.ಎಸ್. ಪ್ರಶೀಲ ಕುಮಾರಿ, ಉಪ ಕಾರ್ಯದರ್ಶಿ (ಅಭಿಪ್ರಾಯ–2)

ಶ್ರೀ ಎಂ. ಮಹಾದೇವಯ್ಯ, ಉಪ ಕಾರ್ಯದರ್ಶಿ (ಅಭಿಪ್ರಾಯ–3)

ಶ್ರೀ ಪಿ. ನರಸಿಂಹಮೂರ್ತಿ,
ಶಾಖಾಧಿಕಾರಿ (ಅಭಿಪ್ರಾಯ)

---

ಶ್ರೀ ಕೆ.ಡಿ.ದೇಶಪಾಂಡೆ
ಅಪರ ಕಾರ್ಯದರ್ಶಿ–1

ಶ್ರೀ ಸುಖದೇವ್ ಮೊನಪ್ಪ ನಾಯಕ್, ಅಪರ ಕಾರ್ಯದರ್ಶಿ–2

ಶ್ರೀ ಎಸ್.ಎಂ.ಶಿವನಗೌಡರ,
ಅಪರ ಕಾರ್ಯದರ್ಶಿ–3

ಶ್ರೀ ಶ್ರೀಧರ ಗೋಪಾಲಕೃಷ್ಣ ಭಟ್, ವಾದೇಕ್ಷಕರು ಹಾಗೂ ಪದನಿಮಿತ್ತ ಸರ್ಕಾರದ ಉಪ ಕಾರ್ಯದರ್ಶಿ(ಪ್ರ)

ಶ್ರೀ ಬಾಲಗೋಪಾಲಕೃಷ್ಣ,
ಸಹಾಯಕ ವಾದೇಕ್ಷಕರು ಹಾಗೂ ಪದನಿಮಿತ್ತ ಅಧೀನ ಕಾರ್ಯದರ್ಶಿ (ವ್ಯಾಜ್ಯ–6)

ಶ್ರೀ ಶ್ರೀಧರ ಗೋಪಾಲಕೃಷ್ಣ ಭಟ್, ಸಹಾಯಕ ವಾದೇಕ್ಷಕರು ಹಾಗೂ ಪದನಿಮಿತ್ತ ಅಧೀನ ಕಾರ್ಯದರ್ಶಿ(ವ್ಯಾಜ್ಯ–7)

ಶ್ರೀ ಅ.ರಾ.ಚಿತ್ತರಗಿ
ಶಾಖಾಧಿಕಾರಿ (ವ್ಯಾಜ್ಯ–6)

ಶ್ರೀಮತಿ ಚಂದ್ರಾವತಿ
ಶಾಖಾಧಿಕಾರಿ (ವ್ಯಾಜ್ಯ–7)

---

ಶ್ರೀ ಕೆ.ನಾರಾಯಣ,
ಸರ್ಕಾರದ ಉಪ ಕಾರ್ಯದರ್ಶಿ(ಆಡಳಿತ–1)

ಶ್ರೀಮತಿ ಆರ್.ರಂಗಮಣಿ,
ಸರ್ಕಾರದ ಉಪ ಕಾರ್ಯದರ್ಶಿ(ಆಡಳಿತ–2)

ಶ್ರೀ ಎಂ.ಪಿ.ನಾಗರಾಜ,
ಸರ್ಕಾರದ ಅಧೀನ ಕಾರ್ಯದರ್ಶಿ(ಆಡಳಿತ–1)

ಶ್ರೀಮತಿ ರುಕ್ಮಿಣಿ ದಿವಾಕರ್
ಸರ್ಕಾರದ ಅಧೀನ ಕಾರ್ಯದರ್ಶಿ(ಆಡಳಿತ–2)

ಶ್ರೀ ಹೆಚ್,ಎನ್.ಪ್ರಭಾಕರ್
ಶಾಖಾಧಿಕಾರಿ(ಆಡಳಿತ–1)

ಶ್ರೀ ಟಿ.ಕೆ.ಲಕ್ಷ್ಮೀನರಸಯ್ಯ
ಶಾಖಾಧಿಕಾರಿ(ಆಡಳಿತ–2)

ಶ್ರೀ ಮುರಳೀಧರ
ಶಾಖಾಧಿಕಾರಿ(ಸ್ವೀಮರ)

**4(1)ಬಿ(*i*) :– ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯ ಸರ್ಕಾರದ ಪ್ರಧಾನ ಕಾರ್ಯದರ್ಶಿಯವರ ಆಪ್ತ ಶಾಖೆಯ ರಚನೆ**




ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯು ಕರ್ನಾಟಕ ಸರ್ಕಾರದ ಸಚಿವಾಲಯದ ಒಂದು ಇಲಾಖೆಯಾಗಿದ್ದು, ವಿಧಾನಸೌಧ, ಬಹುಮಹಡಿ ಕಟ್ಟಡ ಹಾಗೂ ವಿಕಾಸಸೌಧ, ಇಲ್ಲಿ ಕಾರ್ಯ ನಿರ್ವಹಿಸುತ್ತಿದೆ. ಸರ್ಕಾರದ ಪ್ರಧಾನ ಕಾರ್ಯದರ್ಶಿಯವರು ಇಲಾಖಾ ಮುಖ್ಯಸ್ಥರಾಗಿರುತ್ತಾರೆ. ಈ ಇಲಾಖೆಯಲ್ಲಿ ವಿಶೇಷ ಕಾರ್ಯದರ್ಶಿ(ಒಂದು), ಅಪರ ಕಾನೂನು ಕಾರ್ಯದರ್ಶಿ(ನಾಲ್ಕು), ಉಪ ಕಾರ್ಯದರ್ಶಿ(ಏಳು), ಅಧೀನ ಕಾರ್ಯದರ್ಶಿ(ಐದು), ಶಾಖಾಧಿಕಾರಿ(ಎಂಟು) ಅಧಿಕಾರಿಗಳಲ್ಲದೆ ಇತರೆ ವರ್ಗದ ಗ್ರೂಪ್–ಸಿ ಮತ್ತು ಡಿ ವೃಂದದ ನೌಕರರಿರುತ್ತಾರೆ.

ಕರ್ನಾಟಕ ಸರ್ಕಾರದ ಸಚಿವಾಲಯದ ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆ ಈ ಕೆಳಕಾಣಿಸಿರುವ ವಿಭಾಗಗಳನ್ನು ಒಳಗೊಂಡಿದೆ.

1. ಆಡಳಿತ ವಿಭಾಗ
2. ವ್ಯಾಜ್ಯ ವ್ಯವಹಾರಗಳ ವಿಭಾಗ
3. ಅಭಿಪ್ರಾಯ ವಿಭಾಗ
4. ಅಂತರರಾಜ್ಯ ಜಲವಿವಾದ ವಿಭಾಗ
5. ಮಾನವ ಹಕ್ಕುಗಳ ವಿಭಾಗ
6. ಸ್ವೀಕೃತಿ ಮತ್ತು ರವಾನೆ ವಿಭಾಗ

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯಲ್ಲಿ ಕಾರ್ಯ ನಿರ್ವಹಿಸುತ್ತಿರುವ ಅಧಿಕಾರಿಗಳ ವೃಂದ ಬಲವು ಈ ಕೆಳಕಂಡಂತಿದೆ:

| | | | |
|---|---|---|---|
| 1. | ಸರ್ಕಾರದ ಪ್ರಧಾನ ಕಾರ್ಯದರ್ಶಿ | – | ಒಂದು |
| 2. | ಸರ್ಕಾರದ ವಿಶೇಷ ಕಾರ್ಯದರ್ಶಿ (ಅಂರಾಜವಿ) | – | ಒಂದು |
| 3. | ಸರ್ಕಾರದ ಅಪರ ಕಾರ್ಯದರ್ಶಿ(ಅಭಿಪ್ರಾಯ) | – | ಒಂದು |
| 4. | ಸರ್ಕಾರದ ಅಪರ ಕಾರ್ಯದರ್ಶಿ–1 | – | ಒಂದು |
| 5. | ಸರ್ಕಾರದ ಅಪರ ಕಾರ್ಯದರ್ಶಿ–2 | – | ಒಂದು |

| | | | |
|---|---|---|---|
| 6. | ಸರ್ಕಾರದ ಅಪರ ಕಾರ್ಯದರ್ಶಿ–3 | – | ಒಂದು |
| 7. | ಸರ್ಕಾರದ ಉಪ ಕಾರ್ಯದರ್ಶಿ(ಆಡಳಿತ–1) | – | ಒಂದು |
| 8. | ಸರ್ಕಾರದ ಉಪ ಕಾರ್ಯದರ್ಶಿ(ಆಡಳಿತ–2) | – | ಒಂದು |
| 9. | ಸರ್ಕಾರದ ಉಪ ಕಾರ್ಯದರ್ಶಿ (ಅಂರಾಜವಿ) | – | ಒಂದು |
| 10. | ವಾದೇಕ್ಷಕರು ಮತ್ತು ಪದನಿಮಿತ್ತ ಸರ್ಕಾರದ ಉಪ ಕಾರ್ಯದರ್ಶಿ | – | ಒಂದು |
| 11. | ಸರ್ಕಾರದ ಉಪ ಕಾರ್ಯದರ್ಶಿ(ಅಭಿಪ್ರಾಯ–1) | – | ಒಂದು |
| 12. | ಸರ್ಕಾರದ ಉಪ ಕಾರ್ಯದರ್ಶಿ(ಅಭಿಪ್ರಾಯ–2) | – | ಒಂದು |
| 13. | ಸರ್ಕಾರದ ಉಪ ಕಾರ್ಯದರ್ಶಿ(ಅಭಿಪ್ರಾಯ–3) | – | ಒಂದು |
| 14. | ಸಹಾಯಕ ವಾದೇಕ್ಷಕರು ಮತ್ತು ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ (ವ್ಯಾಜ್ಯ–6) | – | ಒಂದು |
| 15. | ಸಹಾಯಕ ವಾದೇಕ್ಷಕರು ಮತ್ತು ಪದನಿಮಿತ್ತ ಸರ್ಕಾರದ ಅಧೀನ ಕಾರ್ಯದರ್ಶಿ (ವ್ಯಾಜ್ಯ–7) | – | ಒಂದು |
| 16. | ಸರ್ಕಾರದ ಅಧೀನ ಕಾರ್ಯದರ್ಶಿ (ಆಡಳಿತ–1) | – | ಒಂದು |
| 17. | ಸರ್ಕಾರದ ಅಧೀನ ಕಾರ್ಯದರ್ಶಿ (ಆಡಳಿತ–2) | – | ಒಂದು |
| 18. | ಸರ್ಕಾರದ ಅಧೀನ ಕಾರ್ಯದರ್ಶಿ (ಮಾನವ ಹಕ್ಕುಗಳು) | – | ಒಂದು |
| 19. | ಶಾಖಾಧಿಕಾರಿಗಳು | – | ಎಂಟು |

ಈ ಇಲಾಖೆಯಲ್ಲಿ ಈ ಕೆಳಗಿನ ಕ್ಷೇತ್ರ ಇಲಾಖೆ:ಸಂಸ್ಥೆಗಳಿಗೆ ಸಂಬಂಧಿಸಿದ ವಿಷಯಗಳನ್ನು ನಿರ್ವಹಿಸಲಾಗುತ್ತಿದೆ:

1) ರಿಜಿಸ್ಟ್ರಾರ್ ಜನರಲ್, ಕರ್ನಾಟಕ ಉಚ್ಚ ನ್ಯಾಯಾಲಯ
2) ಅಡ್ವೋಕೇಟ್ ಜನರಲ್, ಕರ್ನಾಟಕ ಉಚ್ಚ ನ್ಯಾಯಾಲಯ ಕಟ್ಟಡ
3) ಕರ್ನಾಟಕ ನ್ಯಾಯಾಂಗ ಅಕಾಡಮಿ, ಬೆಂಗಳೂರು
4) ಕರ್ನಾಟಕ ರಾಜ್ಯ ಕಾನೂನು ಸೇವಾ ಪ್ರಾಧಿಕಾರ, ಬೆಂಗಳೂರು
5) ಕರ್ನಾಟಕ ಕಾನೂನು ಮತ್ತು ಸಂಸದೀಯ ಸುಧಾರಣೆ ಸಂಸ್ಥೆ, ಬೆಂಗಳೂರು.
6) ಕರ್ನಾಟಕ ಕಾನೂನು ವಿಶ್ವವಿದ್ಯಾಲಯ, ಹುಬ್ಬಳ್ಳಿ
7) ವಿಘ್ನಾನೇಶ್ವರ ಸರ್ಕಾರಿ ಕಾನೂನು ಕಾಲೇಜು, ಮರ್ತೂರು, ಗುಲ್ಬರ್ಗಾ
8) ಕರ್ನಾಟಕ ಕಾನೂನು ಆಯೋಗ, ಬೆಂಗಳೂರು
9) ಕರ್ನಾಟಕ ಮಾನವ ಹಕ್ಕುಗಳ ಆಯೋಗ, ಬೆಂಗಳೂರು

**ಕಾರ್ಯಗಳು ಮತ್ತು ಕರ್ತವ್ಯಗಳು:**

ಸರ್ಕಾರದ ಪ್ರಧಾನ ಕಾರ್ಯದರ್ಶಿಗಳು ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯ ಅಧಿಕೃತ ಮುಖ್ಯಸ್ಥರಾಗಿದ್ದು, ಇಲಾಖಾ ಸಚಿವರ ಸಾಮಾನ್ಯ ಮತ್ತು ವಿಶೇಷ ನಿರ್ದೇಶನಗಳನ್ನು ನಿಯಮಗಳ ಚೌಕಟ್ಟಿನಲ್ಲಿ ಹಾಗೂ ಕರ್ನಾಟಕ ಸರ್ಕಾರಿ(ವ್ಯವಹಾರ ನಿರ್ವಹಣೆ) ನಿಯಮಗಳಿಗೆ ಒಳಪಟ್ಟು ಅಭಿಪ್ರಾಯ, ವ್ಯಾಜ್ಯ, ಆಡಳಿತ ಪ್ರಕರಣಗಳ ವಿಲೇವಾರಿ ಮತ್ತು ವ್ಯವಹಾರದ ಅಂತಿಮ ಜವಾಬ್ದಾರಿ ಹೊಂದಿರುತ್ತಾರೆ. ಪ್ರಧಾನ ಕಾರ್ಯದರ್ಶಿಯವರ ಹುದ್ದೆಗೆ ಪೂರಕ ಸಿಬ್ಬಂದಿ ಆಪ್ತ ಶಾಖೆಯಲ್ಲಿ ಈ ಕೆಳಕಂಡಂತೆ ಕಾರ್ಯ ನಿರ್ವಹಿಸುತ್ತಾರೆ

1. ಪ್ರಧಾನ ಕಾರ್ಯದರ್ಶಿಯವರ ಆಪ್ತ ಶಾಖೆಯಲ್ಲಿ ಸ್ವೀಕರಿಸಲಾಗುವ ಪತ್ರಗಳು ಹಾಗೂ ಕಡತಗಳ ನಿರ್ವಹಣೆ.
2. ಇತರೆ ಇಲಾಖೆಗಳಿಂದ, ಕ್ಷೇತ್ರ ಇಲಾಖೆಗಳಿಂದ ಸ್ವೀಕೃತವಾಗುವ ಪ್ರಸ್ತಾವನೆ / ಪತ್ರಗಳನ್ನು ಪ್ರಧಾನ ಕಾರ್ಯದರ್ಶಿಯವರ ಅನುಮೋದನೆ ನಂತರ ಸಂಬಂಧಪಟ್ಟ ಕಾರ್ಯನಿರತ ವಿಭಾಗ/ಶಾಖೆಗಳಿಗೆ ರವಾನಿಸುವುದು.
3. ಪ್ರಧಾನ ಕಾರ್ಯದರ್ಶಿಯವರು ನೀಡುವ ಉಕ್ತಲೇಖನವನ್ನು ತೆಗೆದುಕೊಂಡು ಅದನ್ನು ಬೆರಳಚ್ಚಿಸಿ ಶುದ್ಧ ಪ್ರತಿಯನ್ನು ಕ್ಷಿಪ್ರವಾಗಿ ನೀಡುವುದು.
4. ಪ್ರಧಾನ ಕಾರ್ಯದರ್ಶಿಯವರ ಕಾರ್ಯಕಲಾಪ, ಸಭೆ/ ಭೇಟಿ ಮುಂತಾದವುಗಳ ಬಗ್ಗೆ ಮಾಹಿತಿ ನಿರ್ವಹಣೆ ಹಾಗೂ ಸಚಿವಾಲಯ ಕೈಪಿಡಿಯಲ್ಲಿ ನಮೂದಿಸಿರುವಂತೆ ಆಪ್ತ ಶಾಖೆಗೆ ವಹಿಸಿರುವ ಇತರೆ ಕಾರ್ಯಗಳು.
5. ಪ್ರಧಾನ ಕಾರ್ಯದರ್ಶಿಯವರ ವೈಯಕ್ತಿಕ ಕಡತ / ಪತ್ರಗಳ ನಿರ್ವಹಣೆ.
6. ಅಧಿಕಾರಿಯವರಿಗೆ ಸಂಬಂಧಪಟ್ಟಂತೆ ಬಿಲ್‌ಗಳನ್ನು ತಯಾರಿಸಿ, ನಿರ್ವಹಿಸುವುದು.
7. ದೂರವಾಣಿ ಕರೆಗಳ ನಿರ್ವಹಣೆ/ ಫ್ಯಾಕ್ಸ್ ನಿರ್ವಹಣೆ.
8. ಕಛೇರಿಗೆ ಅವಶ್ಯವಿರುವ ಲೇಖನ ಸಾಮಗ್ರಿ ಖರೀದಿ, ವಿತರಣೆ ದಾಸ್ತಾನುವಹಿ ನಿರ್ವಹಣೆ.
9. ಪ್ರಧಾನ ಕಾರ್ಯದರ್ಶಿಯವರ ಸಭೆ / ಪರಿಶೀಲನೆ / ಪ್ರವಾಸ / ಪರಿವೀಕ್ಷಣೆ ಇತ್ಯಾದಿ ಸಮನ್ವಯ ಕಾರ್ಯಗಳು.

4(1)ಬಿ(*ii*) :- ಅಧಿಕಾರಿ ಮತ್ತು ನೌಕರರುಗಳ ಹೊಣೆಗಾರಿಕೆ ಮತ್ತು ಕರ್ತವ್ಯಗಳು

| | |
|---|---|
| 1) ಆಪ್ತ ಕಾರ್ಯದರ್ಶಿ : (ಗ್ರೇಡ್–1) | ಸರ್ಕಾರದ ಪ್ರಧಾನ ಕಾರ್ಯದರ್ಶಿಯವರ ಆದೇಶದ ಮೇರೆಗೆ ಉಕ್ತಲೇಖನವನ್ನು ತೆಗೆದುಕೊಂಡು ಅದನ್ನು ಶೀಘ್ರವಾಗಿ ಗಣಕಯಂತ್ರದಲ್ಲಿ ಬೆರಳಚ್ಚಿಸುವುದು. ದೂರವಾಣಿ ಕರೆಗಳನ್ನು ಸ್ವೀಕರಿಸಿ ಪ್ರಧಾನ ಕಾರ್ಯದರ್ಶಿಯವರಿಗೆ ಸಂಪರ್ಕ ಕಲ್ಪಿಸುವುದು. ಸಂದರ್ಶಕರು ಬಂದಾಗ ಭೇಟಿಗೆ ಏರ್ಪಾಡು ಮಾಡುವುದು. ಅಧಿಕಾರಿಗಳ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ನಿಖರವಾದ ಮಾಹಿತಿಗಳನ್ನು ಪಟ್ಟಿ ಮಾಡಿ ಅವುಗಳಿಗೆ ಸಂಬಂಧಿಸಿದ ಟಿಪ್ಪಣಿಗಳನ್ನು ತಯಾರಿಸಿಡುವುದು ಹಾಗೂ ಅವುಗಳನ್ನು ಅನುಸರಿಸುವಂತೆ ಸಕಾಲದಲ್ಲಿ ಅಧಿಕಾರಿಯವರಿಗೆ ನೆನಪು ಮಾಡುವುದು. ಪ್ರಧಾನ ಕಾರ್ಯದರ್ಶಿಯವರಿಂದ ಸೂಚಿಸಲ್ಪಟ್ಟ ಇತರೆ ಕಛೇರಿ ಕೆಲಸಗಳು. ಪ್ರಧಾನ ಕಾರ್ಯದರ್ಶಿಯವರ ಹೆಸರಿನಲ್ಲಿ ಸ್ವೀಕೃತವಾದ ಟಪಾಲುಗಳು ಹಾಗೂ ಕಡತಗಳಲ್ಲಿ ನಿರ್ದೇಶಿಸಲ್ಪಟ್ಟಿರುವ ವಿಷಯಗಳನ್ನು ಕಾರ್ಯರೂಪಕ್ಕೆ ತರುವುದು.<br><br>ಪ್ರಧಾನ ಕಾರ್ಯದರ್ಶಿಯವರ ಅಧೀನದಲ್ಲಿ ಬರುವ ಕಾರ್ಯನಿರತ ವಿಭಾಗಗಳ ವಿಶೇಷ ಕಾರ್ಯದರ್ಶಿ / ಅಪರ ಕಾರ್ಯದರ್ಶಿ / ಉಪ ಕಾರ್ಯದರ್ಶಿಗಳಿಂದ ಸ್ವೀಕೃತವಾಗುವ ಕಡತಗಳನ್ನು ಪ್ರಧಾನ ಕಾರ್ಯದರ್ಶಿಯವರ ಅನುಮೋದನೆಗಾಗಿ ಸಲ್ಲಿಸುವುದು.<br><br>ಪ್ರಧಾನ ಕಾರ್ಯದರ್ಶಿಯವರ ಪ್ರವಾಸ ಕಾರ್ಯಕ್ರಮಗಳನ್ನು ಏರ್ಪಡಿಸುವುದು, ಅದಕ್ಕೆ ಸಂಬಂಧಿಸಿದ ವಿಮಾನ / ರೈಲು ಪ್ರಯಾಣದ ಟಿಕೆಟ್‌ಗಳನ್ನು ಕಾಯ್ದಿರಿಸಿ ಸಕಾಲದಲ್ಲಿ ಒದಗಿಸುವುದು ಹಾಗೂ ಪ್ರಯಾಣ ಭತ್ಯೆಯ ಬಿಲ್‌ಗಳನ್ನು ತಯಾರಿಸುವುದು. ಕಛೇರಿ ಲೇಖನ ಸಾಮಗ್ರಿ ಬಿಲ್, ರಿಫ್ರೆಷ್‌ಮೆಂಟ್ ಬಿಲ್, ವಾಹನದ ಇಂಧನ ಬಿಲ್, ಇತ್ಯಾದಿ ಬಿಲ್‌ಗಳನ್ನು ತಯಾರಿಸಿ ಮಂಜೂರಾತಿಗಾಗಿ ಸಂಬಂಧಿಸಿದ ಇಲಾಖೆಯ ಲೆಕ್ಕಪತ್ರ ವಿಭಾಗಕ್ಕೆ ಕಳುಹಿಸುವುದು. ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಕಾರ್ಯದರ್ಶಿಯವರ ಇನ್ನಿತರೆ ಕೆಲಸಗಳು. |
| 2) ಪತ್ರಾಂಕಿತ ಆಪ್ತ ಸಹಾಯಕರು: | ಸರ್ಕಾರದ ಪ್ರಧಾನ ಕಾರ್ಯದರ್ಶಿಯವರ ಆದೇಶದ ಮೇರೆಗೆ ಉಕ್ತಲೇಖನವನ್ನು ತೆಗದುಕೊಂಡು ಅದನ್ನು ಶೀಘ್ರವಾಗಿ ಗಣಕಯಂತ್ರದಲ್ಲಿ ಬೆರಳಚ್ಚಿಸುವುದು. ದೂರವಾಣಿ ಕರೆಗಳನ್ನು ಸ್ವೀಕರಿಸಿ ಪ್ರಧಾನ ಕಾರ್ಯದರ್ಶಿಯವರಿಗೆ ಸಂಪರ್ಕ ಕಲ್ಪಿಸುವುದು. ಸಂದರ್ಶಕರು ಬಂದಾಗ ಭೇಟಿಗೆ ಏರ್ಪಾಡು ಮಾಡುವುದು. ಅಧಿಕಾರಿಗಳ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ನಿಖರವಾದ ಮಾಹಿತಿಗಳನ್ನು ಪಟ್ಟಿ ಮಾಡಿ ಅವುಗಳಿಗೆ ಸಂಬಂಧಿಸಿದ ಟಿಪ್ಪಣಿಗಳನ್ನು ತಯಾರಿಸಿಡುವುದು ಹಾಗೂ ಅವುಗಳನ್ನು ಅನುಸರಿಸುವಂತೆ ಸಕಾಲದಲ್ಲಿ ಅಧಿಕಾರಿಯವರಿಗೆ ನೆನಪು ಮಾಡುವುದು. ಪ್ರಧಾನ ಕಾರ್ಯದರ್ಶಿಯವರಿಂದ ಸೂಚಿಸಲ್ಪಟ್ಟ ಇತರೆ ಕಛೇರಿ ಕೆಲಸಗಳು. ಪ್ರಧಾನ ಕಾರ್ಯದರ್ಶಿಯವರ ಹೆಸರಿನಲ್ಲಿ ಸ್ವೀಕೃತವಾದ ಟಪಾಲುಗಳು ಹಾಗೂ ಕಡತಗಳಲ್ಲಿ ನಿರ್ದೇಶಿಸಲ್ಪಟ್ಟಿರುವ ವಿಷಯಗಳನ್ನು ಕಾರ್ಯರೂಪಕ್ಕೆ ತರುವುದು. ಹಾಗೂ ಅಧೀನ ಅಧಿಕಾರಿಗಳಿಂದ ಸ್ವೀಕೃತವಾಗುವ ಕಡತಗಳನ್ನು ಪ್ರಧಾನ ಕಾರ್ಯದರ್ಶಿಯವರ ಅನುಮೋದನೆಗಾಗಿ ಸಲ್ಲಿಸುವುದು.<br>ಪ್ರಧಾನ ಕಾರ್ಯದರ್ಶಿಯವರ ಪ್ರವಾಸ ಕಾರ್ಯಕ್ರಮಗಳನ್ನು ಏರ್ಪಡಿಸುವುದು, ಅದಕ್ಕೆ ಸಂಬಂಧಿಸಿದ ವಿಮಾನ / ರೈಲು ಪ್ರಯಾಣದ ಟಿಕೆಟ್‌ಗಳನ್ನು ಕಾಯ್ದಿರಿಸಿ ಸಕಾಲದಲ್ಲಿ ಒದಗಿಸುವುದು ಹಾಗೂ ಪ್ರಯಾಣ ಭತ್ಯೆಯ ಬಿಲ್‌ಗಳನ್ನು ತಯಾರಿಸುವುದು. ಕಛೇರಿ ಲೇಖನ ಸಾಮಗ್ರಿ ಬಿಲ್, ರಿಫ್ರೆಷ್‌ಮೆಂಟ್ ಬಿಲ್, ವಾಹನದ ಇಂಧನ ಬಿಲ್, ಇತ್ಯಾದಿ ಬಿಲ್‌ಗಳನ್ನು ತಯಾರಿಸಿ ಮಂಜೂರಾತಿಗಾಗಿ ಸಂಬಂಧಿಸಿದ ಇಲಾಖೆಯ ಲೆಕ್ಕಪತ್ರ ವಿಭಾಗಕ್ಕೆ ಕಳುಹಿಸುವುದು. ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಕಾರ್ಯದರ್ಶಿಯವರ ಇನ್ನಿತರೆ ಕೆಲಸಗಳು. |
| 3) ಶೀಘ್ರಲಿಪಿಗಾರರು : | ಸರ್ಕಾರದ ಪ್ರಧಾನ ಕಾರ್ಯದರ್ಶಿಯವರ ಆದೇಶದ ಮೇರೆಗೆ ಉಕ್ತಲೇಖನವನ್ನು ತೆಗದುಕೊಂಡು ಅದನ್ನು ಶೀಘ್ರವಾಗಿ ಗಣಕಯಂತ್ರದಲ್ಲಿ ಬೆರಳಚ್ಚಿಸಿ ಸಲ್ಲಿಸುವುದು. ದೂರವಾಣಿ ಕರೆಗಳನ್ನು ಸ್ವೀಕರಿಸಿ ಪ್ರಧಾನ ಕಾರ್ಯದರ್ಶಿಯವರಿಗೆ ಸಂಪರ್ಕ ಕಲ್ಪಿಸುವುದು. ಸಂದರ್ಶಕರು ಬಂದಾಗ ಭೇಟಿಗೆ ಏರ್ಪಾಡು ಮಾಡುವುದು. ಅಧಿಕಾರಿಗಳ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ನಿಖರವಾದ ಮಾಹಿತಿಗಳನ್ನು ಪಟ್ಟಿ ಮಾಡಿ ಅವುಗಳಿಗೆ ಸಂಬಂಧಿಸಿದ ಟಿಪ್ಪಣಿಗಳನ್ನು ತಯಾರಿಸಲು ಆಪ್ತ ಕಾರ್ಯದರ್ಶಿ ಹಾಗೂ ಪತ್ರಾಂಕಿತ ಆಪ್ತ ಸಹಾಯಕರಿಗೆ ಸಹಕರಿಸುವುದು ಹಾಗೂ ಅವುಗಳನ್ನು ಅನುಸರಿಸುವಂತೆ ಸಕಾಲದಲ್ಲಿ ಅಧಿಕಾರಿಯವರಿಗೆ ನೆನಪು ಮಾಡುವುದು. ಪ್ರಧಾನ ಕಾರ್ಯದರ್ಶಿ/ಆಪ್ತ ಕಾರ್ಯದರ್ಶಿಯವರಿಂದ ಸೂಚಿಸಲ್ಪಟ್ಟ ಇತರೆ ಕಛೇರಿ ಕೆಲಸಗಳು. ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಆಪ್ತ ಶಾಖೆಯ ಇನ್ನಿತರೆ ಕೆಲಸಗಳು. |

| | |
|---|---|
| 4) ಕಿರಿಯ ಸಹಾಯಕರು : | ಸರ್ಕಾರದ ಪ್ರಧಾನ ಕಾರ್ಯದರ್ಶಿಯವರಿಗೆ ವಿಳಾಸಿಸಿರುವ ಪತ್ರಗಳನ್ನು / ಕಡತಗಳನ್ನು ಸ್ವೀಕರಿಸಿದ ಕೂಡಲೇ ಸಹಾಯಕರ ವಹಿಯಲ್ಲಿ ನೋಂದಾಯಿಸುವುದು ನಂತರ ರವಾನಿಸುವುದು. ನಿಗದಿತ ತ:ಖ್ತೆಗಳ, ನಿಯತಕಾಲಿಕ ಸವಿವರಣೆಗಳ ತಯಾರಿಕೆ. ಅಧೀನ ಅಧಿಕಾರಿಗಳಿಂದ ಪ್ರಧಾನ ಕಾರ್ಯದರ್ಶಿಯವರಿಗೆ ಬರುವ ಕಡತ ಮತ್ತು ಪತ್ರಗಳನ್ನು ಗಣಕಯಂತ್ರ(ಎಲ್.ಎಂ.ಎಸ್. ಹಾಗೂ ಎಫ್.ಎಂ.ಎಸ್.) ಚಲನವಲನ ನಿರ್ವಹಣೆ. ಮೇಲಧಿಕಾರಿಗಳು ಸೂಚಿಸುವ ಇನ್ನಿತರೆ ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಇನ್ನಿತರೆ ಕೆಲಸಗಳು. |
| 5) ಜಮೇದಾರ್ / ದಲಾಯತ್: | ಕಛೇರಿಯನ್ನು ಅಚ್ಚುಕಟ್ಟಾಗಿ ಚೊಕ್ಕಟವಾಗಿಡುವುದು. ಪ್ರಧಾನ ಕಾರ್ಯದರ್ಶಿಯವರ ಕರೆಗಂಟೆಗೆ ಓಗೊಡುವುದು. ಇತರೆ ಶಾಖೆಗಳಿಗೆ /ಇಲಾಖೆಗಳಿಗೆ ಕಡತಗಳನ್ನು ಹಾಗೂ ಟಪಾಲುಗಳನ್ನು ಖುದ್ದಾಗಿ ತಲುಪಿಸುವುದು. ಕಛೇರಿಯ ಮೇಲಧಿಕಾರಿಗಳು ಸೂಚಿಸುವ ಕೆಲಸಗಳು ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಇನ್ನಿತರೆ ಕೆಲಸಗಳ ಜೊತೆಗೆ ಜೆರಾಕ್ಸ್ ಯಂತ್ರದ ನಿರ್ವಹಣೆ. |
| 6) ವಾಹನ ಚಾಲಕರು : | ಪ್ರಧಾನ ಕಾರ್ಯದರ್ಶಿಯವರ ಕಛೇರಿ ಉಪಯೋಗಕ್ಕಿರುವ ಸರ್ಕಾರದ ಅಧಿಕೃತ ವಾಹನವನ್ನು ನಿರ್ವಹಿಸುವುದು ಹಾಗೂ ಚಾಲಿಸುವುದು. ವಾಹನದ ಲಾಗ್ ಪುಸ್ತಕ ನಿರ್ವಹಣೆ ಹಾಗೂ ವಾಹನವನ್ನು ಸುಸ್ಥಿತಿಯಲ್ಲಿಡುವುದು. ಸಚಿವಾಲಯದ ಕೈಪಿಡಿಯಲ್ಲಿ ಸೂಚಿಸಿರುವಂತೆ ಚಾಲಕರ ಕರ್ತವ್ಯಗಳನ್ನು ನಿರ್ವಹಿಸುವುದು. |

**4(1)ಬಿ(*iii*) :– ಮೇಲ್ವಿಚಾರಣೆ ಮತ್ತು ಹೊಣೆಗಾರಿಕೆಯ ಮಾರ್ಗಗಳು ಸೇರಿದಂತೆ ತೀರ್ಮಾನ ತೆಗೆದುಕೊಳ್ಳುವ ಪ್ರಕ್ರಿಯೆಯಲ್ಲಿ ಅನುಸರಿಸಬೇಕಾದ ಕಾರ್ಯವಿಧಾನ:**

1) ಆಪ್ತ ಕಾರ್ಯದರ್ಶಿ(ಗ್ರೇಡ್–1):– ಪ್ರಧಾನ ಕಾರ್ಯದರ್ಶಿಯವರ ಆಪ್ತ ಕಾರ್ಯದರ್ಶಿಯಾಗಿ ಅವರ ಸಲಹೆ ಹಾಗೂ ಸೂಚನೆಯ ಮೇರೆಗೆ ಆಪ್ತ ಶಾಖೆಯ ಕಛೇರಿ ಕಾರ್ಯಗಳ ಜೊತೆಗೆ ಆಪ್ತ ಶಾಖೆಯ ಮೇಲ್ವಿಚಾರಣೆಯನ್ನು ನಿರ್ವಹಿಸುವುದು.

2) ಪತ್ರಾಂಕಿತ ಆಪ್ತ ಸಹಾಯಕರು:– ಪ್ರಧಾನ ಕಾರ್ಯದರ್ಶಿಯವರ ಪತ್ರಾಂಕಿತ ಆಪ್ತ ಸಹಾಯಕರಾಗಿ ಅವರ ಸಲಹೆ ಹಾಗೂ ಸೂಚನೆಯ ಮೇರೆಗೆ ಆಪ್ತ ಶಾಖೆಯ ಕಛೇರಿ ಕಾರ್ಯಗಳ ಜೊತೆಗೆ ಆಪ್ತ ಶಾಖೆಯ ಮೇಲ್ವಿಚಾರಣೆಯನ್ನು ನಿರ್ವಹಿಸುವುದು.

3) ಶೀಘ್ರಲಿಪಿಗಾರರು:– ಪ್ರಧಾನ ಕಾರ್ಯದರ್ಶಿಯವರ ಆಪ್ತ ಸಹಾಯಕರಾಗಿ ಅವರ ಸಲಹೆ ಹಾಗೂ ಸೂಚನೆಯ ಮೇರೆಗೆ ಬೆರಳಚ್ಚು, ಕಾರ್ಯಕ್ರಮ ಪಟ್ಟಿ ಹಾಗೂ ದಿನಚರಿ ಒಳಗೊಂಡಂತೆ ಆಪ್ತ ಶಾಖೆಯ ಕಛೇರಿ ಕಾರ್ಯಗಳನ್ನು ನಿರ್ವಹಿಸುವುದು.

4) ಕಿರಿಯ ಸಹಾಯಕರು:– ಕರ್ನಾಟಕ ಸರ್ಕಾರ ಸಚಿವಾಲಯ ಕೈಪಿಡಿಯಲ್ಲಿ ಸೂಚಿಸಿರುವಂತೆ ಸರ್ಕಾರದ ಪ್ರಧಾನ ಕಾರ್ಯದರ್ಶಿಯವರಿಗೆ ಬರುವ ಎಲ್ಲಾ ಕಡತಗಳ ಮತ್ತು ಪತ್ರಗಳ ನಿರ್ವಹಣೆ ಹಾಗೂ ಚಲನವಲನ ನಮೂದನ್ನು ಸಂಬಂಧಿಸಿದ ವಹಿಗಳಲ್ಲಿ ನೋಂದಾಯಿಸಿ ಅವುಗಳ ರವಾನೆ ಕಾರ್ಯಗಳನ್ನು ಅಂದಂದೇ ನಿರ್ವಹಿಸುವುದು.

5) ಜಮೇದಾರ್ / ದಲಾಯತ್ :– ಕಛೇರಿಯ ಸಮಯಕ್ಕೆ ಮುಂಚೆಯೇ ಹಾಜರಾಗಿ ಕಛೇರಿಯನ್ನು ಸ್ವಚ್ಛವಾಗಿಡುವುದು. ಕಡತ / ಟಪಾಲುಗಳನ್ನು ಮುಖ್ಯ ಮಂತ್ರಿಯವರ ಕಛೇರಿ / ಮುಖ್ಯ ಕಾರ್ಯದರ್ಶಿಯವರ ಕಛೇರಿ / ಇಲಾಖಾ ಸಚಿವರ ಕಛೇರಿ / ಇತರ ಇಲಾಖಾ ಕಾರ್ಯದರ್ಶಿಗಳ ಕಛೇರಿ ಹಾಗೂ ಸಂಬಂಧಪಟ್ಟ ವಿಭಾಗ / ಶಾಖೆಗಳಿಗೆ ಕೂಡಲೇ ಅಂದಂದೇ ತಲುಪಿಸುವುದು.

**4(1)ಬಿ(*iv*) :– ಕರ್ತವ್ಯ ನಿರ್ವಹಿಸುವಲ್ಲಿ ಅನುಸರಿಸಬೇಕಾದ ಮಾದರಿ/ ಗೊತ್ತುಪಡಿಸಿದ ನಿಗದಿಪಡಿಸಿರುವ ಮಾರ್ಗಸೂಚಿಗಳು:**

2005ರ ಕರ್ನಾಟಕ ಸರ್ಕಾರ ಸಚಿವಾಲಯದ ಪರಿಷ್ಕೃತ ಕೈಪಿಡಿ, ಸಚಿವಾಲಯ ವಾಹಿನಿ ಹಾಗೂ ಕರ್ನಾಟಕ ಸರ್ಕಾರದ(ವ್ಯವಹಾರ ಹಂಚಿಕೆ) ನಿಯಮಗಳು, 1977 ಹಾಗೂ ಕಾಲಕಾಲಕ್ಕೆ ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಗಳಿಂದ ಹೊರಡಿಸಲಾಗುವ ಆದೇಶ, ಇತರೆ ಸರ್ಕಾರಿ ಆದೇಶಗಳು ಮತ್ತು ಸುತ್ತೋಲೆಗಳು

**4(1)ಬಿ(*v*) :– ಸಿಬ್ಬಂದಿ/ಅಧಿಕಾರಿಗಳು ಕರ್ತವ್ಯ ನಿರ್ವಹಣೆಯಲ್ಲಿ ಬಳಸುವ ನಿಯಮಗಳ, ಕಾಯಿದೆಗಳ ಮತ್ತು ಸೂಚನೆಗಳ ಕೈಪಿಡಿಗಳ ವಿವರ:**

1 2005 ಕರ್ನಾಟಕ ಸರ್ಕಾರ ಸಚಿವಾಲಯದ ಪರಿಷ್ಕೃತ ಕೈಪಿಡಿ

2 ಮಾಹಿತಿ ಹಕ್ಕು ಅಧಿನಿಯಮ 2005

3 ಕರ್ನಾಟಕ ನಾಗರೀಕ ಸೇವಾ ನಿಯಮಗಳು 1958

4 ಕರ್ನಾಟಕ ಸಾದಿಲ್ವಾರು ವೆಚ್ಚದ ಕೈಪಿಡಿ, 1958

5 ಕರ್ನಾಟಕ ಸರ್ಕಾರದ(ವ್ಯವಹಾರ ಹಂಚಿಕೆ) ನಿಯಮಗಳು 1977

6 ಕರ್ನಾಟಕ ಸಾರ್ವಜನಿಕ ಸಂಗ್ರಹಣೆಯಲ್ಲಿ ಪಾರದರ್ಶಕತೆ ಅಧಿನಿಯಮ–1999

7 ಕರ್ನಾಟಕ ಸಾರ್ವಜನಿಕ ಸಂಗ್ರಹಣೆಯಲ್ಲಿ ಪಾರದರ್ಶಕತೆ(ತಿದ್ದುಪಡಿ) ಅಧಿನಿಯಮ–2001

8 ಆರ್ಥಿಕ ಇಲಾಖೆಯಿಂದ ಕಾರ್ಯದರ್ಶಿಯವರಿಗೆ ಪ್ರತ್ಯಾಯೋಜಿಸಿರುವ ಆರ್ಥಿಕ ಅಧಿಕಾರದ ಆದೇಶಗಳು.

9 ಕರ್ನಾಟಕ ನ್ಯಾಯಾಂಗ ಅಧಿಕಾರಿಗಳ(ವೈದ್ಯಕೀಯ ಹಾಜರಾತಿ) ನಿಯಮಗಳು 2009

10 ಕರ್ನಾಟಕ ಸರ್ಕಾರಿ ನೌಕರರ(ವೈದ್ಯಕೀಯ ಹಾಜರಾತಿ) ನಿಯಮಗಳು, 1963

11 ಕರ್ನಾಟಕ ನಾಗರೀಕ ಸೇವೆಗಳು(ಸಾಮಾನ್ಯ ನೇಮಕಾತಿ) ನಿಯಮಗಳು, 1977

12 ಕರ್ನಾಟಕ ನಾಗರೀಕ ಸೇವೆಗಳು(ನಡತೆ) ನಿಯಮಗಳು, 1966

13 ಕರ್ನಾಟಕ ನಾಗರೀಕ ಸೇವೆಗಳು(ಸಿ.ಸಿ.ಎ) ನಿಯಮಗಳು, 1957

14 ಕರ್ನಾಟಕ ಆರ್ಥಿಕ ಸಂಹಿತೆ, 1958

15 ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ ಹಾಗೂ ಆರ್ಥಿಕ ಇಲಾಖೆ ಹೊರಡಿಸಿರುವ ಆದೇಶ/ಸುತ್ತೋಲೆ

16 ಕರ್ನಾಟಕ ಕಾನೂನು ಅಧಿಕಾರಿಗಳ(ನೇಮಕಾತಿ ಮತ್ತು ಸೇವಾ ಷರತ್ತುಗಳು) ನಿಯಮಗಳು, 1977

17 ನೋಟರಿ ಅಧಿನಿಯಮ ಮತ್ತು ನಿಯಮಗಳು

18 ದಿ ಕರ್ನಾಟಕ ಕಂಡಕ್ಟ್ ಆಫ್ ಗೌರ್ನಮೆಂಟ್ ಲಿಟಿಗೇಷನ್ ರೂಲ್ಸ್, 1985

**4(1)ಬಿ(*vi*) :– ನಿಯಂತ್ರಣದಲ್ಲಿರುವ ದಸ್ತಾವೇಜುಗಳ ಪ್ರವರ್ಗಗಳ ವಿವರ ಪಟ್ಟಿ:**

ಸಚಿವಾಲಯ ವಾಹಿನಿ ಮೇರೆಗೆ ಸಂಬಂಧಪಟ್ಟ ಶಾಖೆಗಳಲ್ಲಿ ಎಲ್ಲಾ ಕಡತಗಳು ಹಾಗೂ ಹಿಂದೆ ಮುಕ್ತಾಯಗೊಂಡಂತಹ ಪ್ರಮುಖ ಕಡತಗಳು ಲಭ್ಯವಿರುತ್ತದೆ. ಆಪ್ತ ಶಾಖೆಯಲ್ಲಿ ಯಾವುದೇ ಕಡತಗಳನ್ನು ಸೃಜಿಸುವುದಿಲ್ಲ.

**4(1)ಬಿ(*vii*):– ಕಾರ್ಯನೀತಿ ರಚನೆ ಅಥವಾ ಅನುಷ್ಠಾನಕ್ಕೆ ಸಂಬಂಧಿಸಿದಂತೆ ಸಾರ್ವಜನಿಕರೊಡನೆ ಸಮಾಲೋಚಿಸಲು ಅಥವಾ ಅವರ ಪ್ರಾತಿನಿಧ್ಯವಿರುವಂತೆ ಮಾಡಲು ಇರುವ ಯಾವುದೇ ವ್ಯವಸ್ಥೆಯ ವಿವರ:**

ಆಪ್ತ ಶಾಖೆಯಲ್ಲಿ ಈ ತರಹದ ವ್ಯವಸ್ಥೆ ಮಾಡಿಕೊಂಡಿರುವುದಿಲ್ಲ.

**4(1)ಬಿ(*viii*):– ಮಂಡಳಿಗಳು, ಪರಿಷತ್ತುಗಳು, ಸಮಿತಿಗಳು ಅಥವಾ ಅದರ ಭಾಗವಾಗಿ ಅಥವಾ ಅದರ ಸಲಹೆಯ ಉದ್ದೇಶಕ್ಕಾಗಿ ರಚಿತವಾದ ಇಬ್ಬರು ಅಥವಾ ಹೆಚ್ಚು ವ್ಯಕ್ತಿಗಳನ್ನೊಳಗೊಂಡ ಮಂಡಳಿಗಳ, ಪರಿಷತ್ತುಗಳ ಸಮಿತಿಗಳ ಮತ್ತು ಇತರ ನಿಕಾಯಗಳ ಸಭೆಗಳು ಸಾರ್ವಜನಿಕರಿಗೆ ಮುಕ್ತವಾಗಿರುತ್ತವೆಯೋ ಅಥವಾ ಅಂತಹ ಸಭೆಗಳ ನಡವಳಿಗಳು ಸಾರ್ವಜನಿಕರಿಗೆ ದೊರಕುತ್ತವೆಯೋ ಎಂಬುದರ ವಿವರ ಪಟ್ಟಿ:**

ಇದು ಆಪ್ತಶಾಖೆಯಾಗಿರುವುದರಿಂದ ಇಲ್ಲಿ ಮೇಲೆ ಹೇಳಿರುವ ವಿವರಗಳ ಪಟ್ಟಿ ಲಭ್ಯವಿರುವುದಿಲ್ಲ. ಸಾರ್ವಜನಿಕರು ಈ ತರಹದ ಮಾಹಿತಿಗಳನ್ನೇನಾದರೂ ಕೇಳಿದರೆ ಅವರಿಗೆ ಸಂಬಂಧಪಟ್ಟ ಶಾಖೆಗಳನ್ನು ಸಂಪರ್ಕಿಸಲು ತಿಳಿಸಲಾಗುವುದು.

**4(1) ಬಿ (*ix) & (x*):– ಪ್ರಧಾನ ಕಾರ್ಯದರ್ಶಿ ಹಾಗೂ ಆಪ್ತ ಶಾಖೆಯ ನೌಕರರ ಮಾಹಿತಿ ಹಾಗೂ ಪಡೆಯುತ್ತಿರುವ ವೇತನ.**

| ಕ್ರಮ ಸಂಖ್ಯೆ | ಹುದ್ದೆ | ಹೆಸರು<br>ಶ್ರೀ/ಶ್ರೀಮತಿ | ದೂರವಾಣಿ ಸಂಖ್ಯೆ | ಮಾಸಿಕ ವೇತನ |
|---|---|---|---|---|
| 1. | ಸರ್ಕಾರದ ಪ್ರಧಾನ ಕಾರ್ಯದರ್ಶಿ | ಕೆ.ಎನ್.ಫಣೀಂದ್ರ | 22353111<br>22033693 | 1,25,461 |
| 2. | ಆಪ್ತ ಕಾರ್ಯದರ್ಶಿ (ಗ್ರೇಡ್–1) | ಎಸ್.ಜೆ.ಸಿಕ್ವೇರಾ | 22353111<br>22033693 | 54,400 |
| 3. | ಪತ್ರಾಂಕಿತ ಆಪ್ತ ಸಹಾಯಕರು | –ಖಾಲಿ– | 22353111<br>22033693 | - |
| 4. | ಶೀಘ್ರಲಿಪಿಗಾರರು | 1) ಕೆ.ರಕ್ಷಿತ<br>2) ಖೋನಮೀರಸಾಹೇಬ ಎಸ್.ಮುಜಾವರ | 22353111<br>22033693 | 22,230<br>22,230 |
| 5. | ಕಿರಿಯ ಸಹಾಯಕರು | 1) ತಿಪ್ಪೇಶ್.ಎಂ<br>2) ಕೆ.ಇ.ಮಂಜುನಾಥ್ | 22353111<br>22033693 | 16,075<br>16,075 |
| 6. | ಜಮೇದಾರ್ | ಎಂ.ಸುಬ್ಬ | 22353111<br>22033693 | 21,750 |

| ಕ್ರಮ ಸಂಖ್ಯೆ | ಹುದ್ದೆ | ಹೆಸರು ಶ್ರೀ/ಶ್ರೀಮತಿ | ದೂರವಾಣಿ ಸಂಖ್ಯೆ | ಮಾಸಿಕ ವೇತನ |
|---|---|---|---|---|
| 7. | ದಲಾಯತ್ | ಕೊಂಡೂರಪ್ಪ ನಾರಾಯಣಪ್ಪ | 22353111<br>22033693 | 15,691 |
| 8. | ವಾಹನ ಚಾಲಕರು | ಕೆ.ವಿಜಯಕುಮಾರ್ | 22353111<br>22033693 | 20,605 |

**4(1) ಬಿ (*xi*):– ಎಲ್ಲಾ ಯೋಜನೆಗಳ ವಿವರಗಳನ್ನು ಸೂಚಿಸುವ ಪ್ರಸ್ತಾವಿತ ವೆಚ್ಚಗಳನ್ನು ಮತ್ತು ಮಾಡಲಾದ ಬಟವಾಡೆಗಳ ವರದಿಯನ್ನು ಸೂಚಿಸಿ ಅದರ ಪ್ರತಿಯೊಂದು ಏಜೆನ್ಸಿಗೆ ಹಂಚಿಕೆ ಮಾಡಲಾದ ಆಯವ್ಯಯ.**

ಇದು ಪ್ರಧಾನ ಕಾರ್ಯದರ್ಶಿಯವರ ಆಪ್ತಶಾಖೆ ಆಗಿರುವುದರಿಂದ ಮೇಲೆ ಹೇಳಿರುವ ಕಾರ್ಯಗಳು ಸಂಬಂಧಪಡುವುದಿಲ್ಲ.

**4(1) ಬಿ (*xii*):– ಹಂಚಿಕೆ ಮಾಡಲಾದ ಮೊಬಲಗುಗಳನ್ನೊಳಗೊಂಡು, ಸಹಾಯ ಧನ ಕಾರ್ಯಕ್ರಮಗಳನ್ನು ಜಾರಿಯ ವಿಧಾನವನ್ನು ಮತ್ತು ಅಂತಹ ಕಾರ್ಯಕ್ರಮಗಳ ಫಲಾನುಭವಿಗಳ ವಿವರ:**

ಇದು ಆಪ್ತಶಾಖೆ ಆಗಿರುವುದರಿಂದ ಮೇಲೆ ಹೇಳಿರುವ ಕಾರ್ಯಗಳು ಸಂಬಂಧಪಡುವುದಿಲ್ಲ.

**4(1) ಬಿ (*xiii*):– ರಿಯಾಯಿತಿಗಳನ್ನು ಪಡೆಯುವವರ, ಅನುಮತಿಗಳು ಅಥವಾ ಸಾರ್ವಜನಿಕ ಪ್ರಾಧಿಕಾರದಿಂದ ಮಂಜೂರಾದ ಅಧಿಕಾರ ಪತ್ರಗಳ ವಿವರಗಳು:**

"ಅನ್ವಯಿಸುವುದಿಲ್ಲ"

**4(1) ಬಿ (*xiv*):- ವಿದ್ಯುನ್ಮಾನ ರೂಪದಲ್ಲಿ ಲಭ್ಯವಿರುವ ಇಲಾಖೆಯ ವಿವಿಧ ಯೋಜನೆಗಳ ವಿವರಗಳು ಮಾಹಿತಿಯನ್ನು ಒದಗಿಸುವುದು(ಫ್ಲಾಪಿ, ಸಿಡಿ, ವಿಸಿಡಿ, ವೆಬ್‌ಸೈಟ್ ಇಂಟರ್‌ನೆಟ್ ಇತ್ಯಾದಿ)**

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಗೆ ಸಂಬಂಧಪಟ್ಟ ಮಾಹಿತಿಗಳು ಇಲಾಖೆಯ ವೆಬ್‌ಸೈಟ್ www.karunadu.gov.in/law/pages/home.aspx ನಲ್ಲಿ ಲಭ್ಯವಿರುತ್ತದೆ.

**4(1) ಬಿ (*xv*):– ಮಾಹಿತಿಯನ್ನು ಪಡೆಯಲು ನಾಗರೀಕರಿಗೆ ಲಭ್ಯವಿರುವ ಸೌಲಭ್ಯಗಳ ಬಗ್ಗೆ ವಿವರಗಳು.**

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಗೆ ಸಂಬಂಧಪಟ್ಟ ಮಾಹಿತಿಗಳು ಇಲಾಖೆಯ ವೆಬ್‌ಸೈಟ್ www.karunadu.gov.in/law/pages/home.aspx ನಲ್ಲಿ ನಾಗರೀಕರು ಪಡೆದುಕೊಳ್ಳಬಹುದು. ಹಾಗೂ ಕರ್ನಾಟಕ ಮಾಹಿತಿ ಹಕ್ಕು ಕಾಯ್ದೆಯನ್ವಯ ಇಲಾಖೆಯ ವತಿಯಿಂದ ನೇಮಕಗೊಂಡ ಮಾಹಿತಿ ಅಧಿಕಾರಿಗಳ ಮೂಲಕ ಮಾಹಿತಿಗಳನ್ನು ಪಡೆದುಕೊಳ್ಳಬಹುದು.

**4(1) ಬಿ (*xvi*):– ಸಾರ್ವಜನಿಕರಿಗೆ ಮಾಹಿತಿ ಅಧಿಕಾರಿಗಳ ಹೆಸರುಗಳು, ಪದನಾಮಗಳು ಮತ್ತು ಇತರೆ ಮಾಹಿತಿ:**

ಇದು ಆಪ್ತಶಾಖೆ ಆಗಿರುವುದರಿಂದ ಸಂಬಂಧಪಟ್ಟ ಮಾಹಿತಿಯನ್ನು ಆಯಾ ಶಾಖೆಗಳಿಂದ ಪಡೆಯಬಹುದು.

**4(1) ಬಿ (*xvii*):– ನಿಯಮಿಸಬಹುದಾದಂತಹ ಮಾಹಿತಿಗಳನ್ನು ಪ್ರಕಟಿಸತಕ್ಕದ್ದು ಮತ್ತು ಆ ತರುವಾಯ ಪ್ರತಿವರ್ಷ ಈ ಪ್ರಕಟಣೆಗಳನ್ನು ಅಂದಿನವರೆಗೆ ಪರಿಷ್ಕರಿಸತಕ್ಕದ್ದು:**

ಅನ್ವಯಿಸುವುದಿಲ್ಲ.

**4(1)ಬಿ(*i*) : ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯ ಸರ್ಕಾರದ ವಿಶೇಷ ಕಾರ್ಯದರ್ಶಿ (ಅಂತರರಾಜ್ಯ ಜಲವಿವಾದ) ರವರ ಆಪ್ತ ಶಾಖೆಯ ರಚನೆ**



**ಕಾರ್ಯಗಳು ಮತ್ತು ಕರ್ತವ್ಯಗಳು:**

ಕಾವೇರಿ ಜಲವಿವಾದ, ಕೃಷ್ಣ ಜಲವಿವಾದ ಮತ್ತು ಮಹದಾಯಿ ಜಲವಿವಾದ ವಿಷಯಗಳು ಮತ್ತು ಹೊರ ರಾಜ್ಯಗಳ ಉಚ್ಚ ನ್ಯಾಯಾಲಯ, ಸರ್ವೋಚ್ಚ ನ್ಯಾಯಾಲಯ, ವಿಶೇಷ ನ್ಯಾಯಾಲಯ, ಇಲ್ಲಿ ಬಾಕಿ ಇರುವ ಪ್ರಕರಣಗಳನ್ನು ನಿರ್ವಹಿಸುವುದು. ಇದಲ್ಲದೆ ರಾಜ್ಯ ಮಾನವ ಹಕ್ಕುಗಳ ಆಯೋಗ, ಕಾನೂನು ಆಯೋಗ, ಕರ್ನಾಟಕ ರಾಜ್ಯ ಕಾನೂನು ವಿಶ್ವವಿದ್ಯಾಲಯ ಮತ್ತು ವಿಘ್ನಾನೇಶ್ವರ ಸರ್ಕಾರಿ ಕಾನೂನು ಕಾಲೇಜು, ಮರ್ತೂರು, ಗುಲ್ಬರ್ಗಾಗೆ ಸಂಬಂಧಿಸಿದ ವಿಷಯಗಳ ನಿರ್ವಹಣೆಯ ಜವಾಬ್ದಾರಿ ಹೊಂದಿರುತ್ತಾರೆ.

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯ ಅಂತರರಾಜ್ಯ ಜಲವಿವಾದ ಮತ್ತು ಮಾನವ ಹಕ್ಕುಗಳ ಶಾಖೆಗಳ ಆಡಳಿತಾತ್ಮಕ ವಿಷಯಗಳಿಗೆ ಸಂಬಂಧಿಸಿದ ವಿಶೇಷ ಕಾರ್ಯದರ್ಶಿ (ಅಂರಾಜವಿ) ರವರ ಹುದ್ದೆಗೆ ಪೂರಕ ಸಿಬ್ಬಂದಿ ಈ ಆಪ್ತ ಶಾಖೆಯಲ್ಲಿ ಈ ಕೆಳಕಂಡ ಕಾರ್ಯನಿರ್ವಹಿಸುತ್ತಾರೆ.

1. ಪ್ರಧಾನ ಕಾರ್ಯದರ್ಶಿಯವರ ಆಪ್ತ ಶಾಖೆಯಿಂದ ಹಾಗೂ ಸಂಬಂಧಪಟ್ಟ ಕ್ಷೇತ್ರ ಇಲಾಖೆಗಳಿಂದ ಸ್ವೀಕರಿಸಲಾಗುವ ಪತ್ರಗಳು ಹಾಗೂ ಕಡತಗಳ ನಿರ್ವಹಣೆ.
2. ಅಧೀನಾಧಿಕಾರಿಯವರಿಂದ ಸ್ವೀಕೃತವಾಗುವ ಪ್ರಸ್ತಾವನೆಗಳನ್ನು ವಿಶೇಷ ಕಾರ್ಯದರ್ಶಿ (ಅಂರಾಜವಿ)ಯವರ ಪರಿಶೀಲನೆ ನಂತರ ಸಂಬಂಧಪಟ್ಟ ವಿಭಾಗಗಳಿಗೆ/ ಶಾಖೆಗಳಿಗೆ ರವಾನಿಸುವುದು.
3. ವಿಶೇಷ ಕಾರ್ಯದರ್ಶಿಯವರು ನೀಡಿದ ಉಕ್ತಲೇಖನವನ್ನು ಶೀಘ್ರಲಿಪಿಯಲ್ಲಿ ಬರೆದುಕೊಳ್ಳುವುದು ಹಾಗೂ ಅದನ್ನು ಸಂಬಂಧಪಟ್ಟ ಕಡತದಲ್ಲಿ ದಾಖಲಿಸಿ ನೀಡುವುದು.
4. ಅಧಿಕಾರಿಯ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ಮಾಹಿತಿ ನಿರ್ವಹಣೆ.
5. ಆಪ್ತ ಶಾಖೆಗೆ ಸಚಿವಾಲಯ ಕೈಪಿಡಿಯಲ್ಲಿ ವಹಿಸಿರುವ ಇತರೆ ಕಾರ್ಯಗಳು.

**4(1)ಬಿ(*ii*) :– ಅಧಿಕಾರಿ ಮತ್ತು ನೌಕರರುಗಳ ಹೊಣೆಗಾರಿಕೆ ಮತ್ತು ಕರ್ತವ್ಯಗಳು**

| | |
|---|---|
| 1) ಶೀಘ್ರಲಿಪಿಗಾರರು : | ಸರ್ಕಾರದ ವಿಶೇಷ ಕಾರ್ಯದರ್ಶಿಯವರ ಆದೇಶದ ಮೇರೆಗೆ ಉಕ್ತಲೇಖನವನ್ನು ತೆಗದುಕೊಂಡು ಅದನ್ನು ಶೀಘ್ರವಾಗಿ ಗಣಕಯಂತ್ರದಲ್ಲಿ ಬೆರಳಚ್ಚಿಸಿ ಸಲ್ಲಿಸುವುದು. ದೂರವಾಣಿ ಕರೆಗಳನ್ನು ಸ್ವೀಕರಿಸಿ ವಿಶೇಷ ಕಾರ್ಯದರ್ಶಿಯವರಿಗೆ ಸಂಪರ್ಕ ಕಲ್ಪಿಸುವುದು. ಸಂದರ್ಶಕರು ಬಂದಾಗ ಭೇಟಿಗೆ ಏರ್ಪಾಡು ಮಾಡುವುದು. ಅಧಿಕಾರಿಗಳ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ನಿಖರವಾದ ಮಾಹಿತಿಗಳನ್ನು ಪಟ್ಟಿ ಮಾಡಿ ಅವುಗಳನ್ನು ಅನುಸರಿಸುವಂತೆ ಸಕಾಲದಲ್ಲಿ ಅಧಿಕಾರಿಯವರಿಗೆ ನೆನಪು ಮಾಡುವುದು. ವಿಶೇಷ ಕಾರ್ಯದರ್ಶಿಯವರಿಂದ ಸೂಚಿಸಲ್ಪಟ್ಟ ಇತರೆ ಕಛೇರಿ ಕೆಲಸಗಳು. ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಆಪ್ತ ಶಾಖೆಯ ಇನ್ನಿತರೆ ಕೆಲಸಗಳು.<br>ವಿಶೇಷ ಕಾರ್ಯದರ್ಶಿಯವರ ಅಧೀನದಲ್ಲಿ ಬರುವ ಕಾರ್ಯನಿರತ ವಿಭಾಗಗಳ ಉಪ ಕಾರ್ಯದರ್ಶಿ / ಅಧೀನ ಕಾರ್ಯದರ್ಶಿಗಳಿಂದ ಸ್ವೀಕೃತವಾಗುವ ಕಡತಗಳನ್ನು ವಿಶೇಷ ಕಾರ್ಯದರ್ಶಿಯವರ ಅನುಮೋದನೆಗಾಗಿ ಸಲ್ಲಿಸುವುದು. |
| 2) ಕಿರಿಯ ಸಹಾಯಕರು : | ಸರ್ಕಾರದ ವಿಶೇಷ ಕಾರ್ಯದರ್ಶಿಯವರಿಗೆ ವಿಳಾಸಿಸಿರುವ ಪತ್ರಗಳನ್ನು / ಕಡತಗಳನ್ನು ಸ್ವೀಕರಿಸಿದ ಕೂಡಲೇ ಸಹಾಯಕರ ವಹಿಯಲ್ಲಿ ನೋಂದಾಯಿಸುವುದು ನಂತರ ರವಾನಿಸುವುದು. ನಿಗದಿತ ತ:ಖ್ತೆಗಳ, ನಿಯತಕಾಲಿಕ ಸವಿವರಣೆಗಳ ತಯಾರಿಕೆ. ಅಧೀನ ಅಧಿಕಾರಿಗಳಿಂದ ವಿಶೇಷ ಕಾರ್ಯದರ್ಶಿಯವರಿಗೆ ಬರುವ ಕಡತ ಮತ್ತು ಪತ್ರಗಳನ್ನು ಗಣಕಯಂತ್ರ(ಎಲ್.ಎಂ.ಎಸ್. ಹಾಗೂ ಎಫ್.ಎಂ.ಎಸ್.) ಚಲನವಲನ ನಿರ್ವಹಣೆ. ಮೇಲಧಿಕಾರಿಗಳು ಸೂಚಿಸುವ ಇನ್ನಿತರೆ ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಇನ್ನಿತರೆ ಕೆಲಸಗಳು. |
| 3) ದಲಾಯತ್ : | ಕಛೇರಿಯನ್ನು ಅಚ್ಚುಕಟ್ಟಾಗಿ ಚೊಕ್ಕಟವಾಗಿಡುವುದು. ವಿಶೇಷ ಕಾರ್ಯದರ್ಶಿಯವರ ಕರೆಗಂಟೆಗೆ ಓಗೊಡುವುದು. ಇತರೆ ಶಾಖೆಗಳಿಗೆ /ಇಲಾಖೆಗಳಿಗೆ ಕಡತಗಳನ್ನು ಹಾಗೂ ಟಪಾಲುಗಳನ್ನು ಖುದ್ದಾಗಿ ತಲುಪಿಸುವುದು. ಕಛೇರಿಯ ಮೇಲಧಿಕಾರಿಗಳು ಸೂಚಿಸುವ ಕೆಲಸಗಳು ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಇನ್ನಿತರೆ ಕೆಲಸಗಳ ಜೊತೆಗೆ ಜೆರಾಕ್ಸ್ ಯಂತ್ರದ ನಿರ್ವಹಣೆ. |

| | |
|---|---|
| 4)ವಾಹನ ಚಾಲಕರು : | ವಿಶೇಷ ಕಾರ್ಯದರ್ಶಿಯವರ ಕಛೇರಿ ಉಪಯೋಗಕ್ಕಿರುವ ಸರ್ಕಾರದ ಅಧಿಕೃತ ವಾಹನವನ್ನು ನಿರ್ವಹಿಸುವುದು ಹಾಗೂ ಚಾಲಿಸುವುದು. ವಾಹನದ ಲಾಗ್ ಪುಸ್ತಕ ನಿರ್ವಹಣೆ ಹಾಗೂ ವಾಹನವನ್ನು ಸುಸ್ಥಿತಿಯಲ್ಲಿಡುವುದು. ಸಚಿವಾಲಯದ ಕೈಪಿಡಿಯಲ್ಲಿ ಸೂಚಿಸಿರುವಂತೆ ಚಾಲಕರ ಕರ್ತವ್ಯಗಳನ್ನು ನಿರ್ವಹಿಸುವುದು. |

**4(1)ಬಿ(*iii*) :- ಮೇಲ್ವಿಚಾರಣೆ ಮತ್ತು ಹೊಣೆಗಾರಿಕೆಯ ಮಾರ್ಗಗಳು ಸೇರಿದಂತೆ ತೀರ್ಮಾನ ತೆಗೆದುಕೊಳ್ಳುವ ಪ್ರಕ್ರಿಯೆಯಲ್ಲಿ ಅನುಸರಿಸಬೇಕಾದ ಕಾರ್ಯವಿಧಾನ:**

1. ಶೀಘ್ರಲಿಪಿಗಾರರು:- ವಿಶೇಷ ಕಾರ್ಯದರ್ಶಿಯವರ ಆಪ್ತ ಸಹಾಯಕರಾಗಿ ಅವರ ಸಲಹೆ ಹಾಗೂ ಸೂಚನೆಯ ಮೇರೆಗೆ ಬೆರಳಚ್ಚು, ಕಾರ್ಯಕ್ರಮ ಪಟ್ಟಿ ಹಾಗೂ ದಿನಚರಿ ಒಳಗೊಂಡಂತೆ ಆಪ್ತ ಶಾಖೆಯ ಕಛೇರಿ ಕಾರ್ಯಗಳನ್ನು ನಿರ್ವಹಿಸುವುದು.
2. ಕಿರಿಯ ಸಹಾಯಕರು:- ಕರ್ನಾಟಕ ಸರ್ಕಾರ ಸಚಿವಾಲಯ ಕೈಪಿಡಿಯಲ್ಲಿ ಸೂಚಿಸಿರುವಂತೆ ಸರ್ಕಾರದ ವಿಶೇಷ ಕಾರ್ಯದರ್ಶಿಯವರಿಗೆ ಬರುವ ಎಲ್ಲಾ ಕಡತಗಳ ಮತ್ತು ಪತ್ರಗಳ ನಿರ್ವಹಣೆ ಹಾಗೂ ಚಲನವಲನ ನಮೂದನ್ನು ಸಂಬಂಧಿಸಿದ ವಹಿಗಳಲ್ಲಿ ನೋಂದಾಯಿಸಿ ಅವುಗಳ ರವಾನೆ ಕಾರ್ಯಗಳನ್ನು ಅಂದಂದೇ ನಿರ್ವಹಿಸುವುದು.
3. ದಲಾಯತ್ :- ಕಛೇರಿಯ ಸಮಯಕ್ಕೆ ಮುಂಚೆಯೇ ಹಾಜರಾಗಿ ಕಛೇರಿಯನ್ನು ಸ್ವಚ್ಛವಾಗಿಡುವುದು. ಕಡತ / ಟಪಾಲುಗಳನ್ನು ಸಂಬಂಧಪಟ್ಟ ವಿಭಾಗ / ಶಾಖೆಗಳಿಗೆ ಕೂಡಲೇ ಅಂದಂದೇ ತಲುಪಿಸುವುದು.

**4(1)ಬಿ(*iv*) :- ಕರ್ತವ್ಯ ನಿರ್ವಹಿಸುವಲ್ಲಿ ಅನುಸರಿಸಬೇಕಾದ ಮಾದರಿ/ ಗೊತ್ತುಪಡಿಸಿದ ನಿಗದಿಪಡಿಸಿರುವ ಮಾರ್ಗಸೂಚಿಗಳು:**

2005ರ ಕರ್ನಾಟಕ ಸರ್ಕಾರ ಸಚಿವಾಲಯದ ಪರಿಷ್ಕೃತ ಕೈಪಿಡಿ, ಸಚಿವಾಲಯ ವಾಹಿನಿ ಹಾಗೂ ಕರ್ನಾಟಕ ಸರ್ಕಾರದ(ವ್ಯವಹಾರ ಹಂಚಿಕೆ) ನಿಯಮಗಳು, 1977, ಮಾನವ ಸಂರಕ್ಷಣಾ ಅಧಿನಿಯಮ 1993(ಕರ್ನಾಟಕ ಕಾಯ್ದೆ ಸಂಖ್ಯೆ:10/1994), ಕರ್ನಾಟಕ ರಾಜ್ಯ ಕಾನೂನು ವಿಶ್ವವಿದ್ಯಾಲಯ ಅಧಿನಿಯಮ, 2009 ಹಾಗೂ ಕಾಲಕಾಲಕ್ಕೆ ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಗಳಿಂದ ಹೊರಡಿಸಲಾಗುವ ಆದೇಶ, ಇತರೆ ಸರ್ಕಾರಿ ಆದೇಶಗಳು ಮತ್ತು ಸುತ್ತೋಲೆಗಳು.

**4(1)ಬಿ(*v*) :- ಸಿಬ್ಬಂದಿ/ಅಧಿಕಾರಿಗಳು ಕರ್ತವ್ಯ ನಿರ್ವಹಣೆಯಲ್ಲಿ ಬಳಸುವ ನಿಯಮಗಳ, ಕಾಯಿದೆಗಳ ಮತ್ತು ಸೂಚನೆಗಳ ಕೈಪಿಡಿಗಳ ವಿವರ:**

| | |
|---|---|
| 1 | 2005 ಕರ್ನಾಟಕ ಸರ್ಕಾರ ಸಚಿವಾಲಯದ ಪರಿಷ್ಕೃತ ಕೈಪಿಡಿ |
| 2 | ಮಾಹಿತಿ ಹಕ್ಕು ಅಧಿನಿಯಮ 2005 |
| 3 | ಕರ್ನಾಟಕ ನಾಗರೀಕ ಸೇವಾ ನಿಯಮಗಳು 1958 |
| 4 | ಕರ್ನಾಟಕ ಸಾದಿಲ್ವಾರು ವೆಚ್ಚದ ಕೈಪಿಡಿ, 1958 |
| 5 | ಕರ್ನಾಟಕ ಸರ್ಕಾರದ (ವ್ಯವಹಾರ ಹಂಚಿಕೆ) ನಿಯಮಗಳು 1977 |
| 6 | ಕರ್ನಾಟಕ ಸರ್ಕಾರದ (ವ್ಯವಹಾರ ನಿರ್ವಹಣೆ) ನಿಯಮಗಳು 1977 |
| 7 | ಕರ್ನಾಟಕ ನಾಗರೀಕ ಸೇವೆಗಳು (ಸಿ.ಸಿ.ಎ) ನಿಯಮಗಳು, 1957 |
| 8 | ಕರ್ನಾಟಕ ಆರ್ಥಿಕ ಸಂಹಿತೆ, 1958 |
| 9 | ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ ಹಾಗೂ ಆರ್ಥಿಕ ಇಲಾಖೆ ಹೊರಡಿಸಿರುವ ಆದೇಶ / ಸುತ್ತೋಲೆ |
| 10 | ದಿ ಕರ್ನಾಟಕ ಕಂಡಕ್ಟ್ ಆಫ್ ಗೌರ್‍ನಮೆಂಟ್ ಲಿಟಿಗೇಷನ್ ರೂಲ್ಸ್, 1985 |
| 11 | ಕೇಂದ್ರದ ಹಾಗೂ ರಾಜ್ಯದ ಇತರೆ ಸಂಬಂಧಿತ ಕಾಯ್ದೆ ಹಾಗೂ ನಿಯಮಗಳು |
| 12 | ಕರ್ನಾಟಕ ರಾಜ್ಯ ವಿಶ್ವವಿದ್ಯಾಲಯ ವಿಧೇಯಕ, 2009 |
| 13 | ಕರ್ನಾಟಕ ಖಜಾನೆ ಸಂಹಿತೆ. |
| 14 | ಮಾನವ ಸಂರಕ್ಷಣಾ ಅಧಿನಿಯಮ, 1993 (ಕರ್ನಾಟಕ ಕಾಯ್ದೆ ಸಂಖ್ಯೆ:10/1994) |

**4(1)ಬಿ(*vi*) :– ನಿಯಂತ್ರಣದಲ್ಲಿರುವ ದಸ್ತಾವೇಜುಗಳ ಪ್ರವರ್ಗಗಳ ವಿವರ ಪಟ್ಟಿ:**

ಸಚಿವಾಲಯ ವಾಹಿನಿ ಮೇರೆಗೆ ಸಂಬಂಧಪಟ್ಟ ಶಾಖೆಗಳಲ್ಲಿ ಎಲ್ಲಾ ಕಡತಗಳು ಹಾಗೂ ಹಿಂದೆ ಮುಕ್ತಾಯಗೊಂಡಂತಹ ಪ್ರಮುಖ ಕಡತಗಳು ಲಭ್ಯವಿರುತ್ತದೆ.

ಆಪ್ತ ಶಾಖೆಯಲ್ಲಿ ಯಾವುದೇ ಕಡತಗಳನ್ನು ಸೃಜಿಸುವುದಿಲ್ಲ. ಗೌಪ್ಯ ಹಾಗೂ ಇತರೆ ಮುಖ್ಯ ಕಡತಗಳನ್ನು ಮಾತ್ರ ಸೃಜಿಸಲಿದ್ದು, ಅವುಗಳನ್ನು ಮಾತ್ರ ನಿರ್ವಹಿಸಲಾಗುವುದು.

**4(1)ಬಿ(*vii*):– ಕಾರ್ಯನೀತಿ ರಚನೆ ಅಥವಾ ಅನುಷ್ಠಾನಕ್ಕೆ ಸಂಬಂಧಿಸಿದಂತೆ ಸಾರ್ವಜನಿಕರೊಡನೆ ಸಮಾಲೋಚಿಸಲು ಅಥವಾ ಅವರ ಪ್ರಾತಿನಿಧ್ಯವಿರುವಂತೆ ಮಾಡಲು ಇರುವ ಯಾವುದೇ ವ್ಯವಸ್ಥೆಯ ವಿವರ:**

ಆಪ್ತ ಶಾಖೆಯಲ್ಲಿ ಈ ತರಹದ ವ್ಯವಸ್ಥೆಯನ್ನು ಮಾಡಿಕೊಂಡಿರುವುದಿಲ್ಲ.

**4(1)ಬಿ(*viii*):– ಮಂಡಳಿಗಳು, ಪರಿಷತ್ತುಗಳು, ಸಮಿತಿಗಳು ಅಥವಾ ಅದರ ಭಾಗವಾಗಿ ಅಥವಾ ಅದರ ಸಲಹೆಯ ಉದ್ದೇಶಕ್ಕಾಗಿ ರಚಿತವಾದ ಇಬ್ಬರು ಅಥವಾ ಹೆಚ್ಚು ವ್ಯಕ್ತಿಗಳನ್ನೊಳಗೊಂಡ ಮಂಡಳಿಗಳ, ಪರಿಷತ್ತುಗಳ ಸಮಿತಿಗಳ ಮತ್ತು ಇತರ ನಿಕಾಯಗಳ ಸಭೆಗಳು ಸಾರ್ವಜನಿಕರಿಗೆ ಮುಕ್ತವಾಗಿರುತ್ತವೆಯೋ ಅಥವಾ ಅಂತಹ ಸಭೆಗಳ ನಡವಳಿಗಳು ಸಾರ್ವಜನಿಕರಿಗೆ ದೊರಕುತ್ತವೆಯೋ ಎಂಬುದರ ವಿವರ ಪಟ್ಟಿ:**

ಇದು ಆಪ್ತಶಾಖೆಯಾಗಿರುವುದರಿಂದ ಇಲ್ಲಿ ಮೇಲೆ ಹೇಳಿರುವ ವಿವರಗಳ ಪಟ್ಟಿ ಲಭ್ಯವಿರುವುದಿಲ್ಲ. ಸಾರ್ವಜನಿಕರು ಈ ತರಹದ ಮಾಹಿತಿಗಳನ್ನೇನಾದರೂ ಕೇಳಿದರೆ ಅವರಿಗೆ ಸಂಬಂಧಪಟ್ಟ ಶಾಖೆಗಳನ್ನು ಸಂಪರ್ಕಿಸಲು ತಿಳಿಸಲಾಗುವುದು.

**4(1) ಬಿ (*ix) & (x*):– ವಿಶೇಷ ಕಾರ್ಯದರ್ಶಿ(ಅಂರಾಜವಿ) ಹಾಗೂ ಆಪ್ತ ಶಾಖೆಯ ನೌಕರರ ಮಾಹಿತಿ ಹಾಗೂ ಪಡೆಯುತ್ತಿರುವ ವೇತನ.**

| ಕ್ರಮ ಸಂಖ್ಯೆ | ಹುದ್ದೆ | ಹೆಸರು ಶ್ರೀ/ಶ್ರೀಮತಿ | ದೂರವಾಣಿ ಸಂಖ್ಯೆ | ಮಾಸಿಕ ವೇತನ |
|---|---|---|---|---|
| 1. | ಸರ್ಕಾರದ ವಿಶೇಷ ಕಾರ್ಯದರ್ಶಿ (ಅಂರಾಜವಿ) | ಕೆ.ಜಿ.ವಿ.ಮೂರ್ತಿ | 22353110 | 81,400 |
| 2. | ಶೀಘ್ರಲಿಪಿಗಾರರು | ಸುನೀತಾ ಆರ್.ಬೇದರೆ | 22353110 | 25,115 |
| 3. | ದಲಾಯತ್ | –ಖಾಲಿ– | - | - |
| 4. | ವಾಹನ ಚಾಲಕರು | ಬಾಬು ಬಾಸ್ಕರ್ | - | 34,250 |

**4(1) ಬಿ (*xi*):– ಎಲ್ಲಾ ಯೋಜನೆಗಳ ವಿವರಗಳನ್ನು ಸೂಚಿಸುವ ಪ್ರಸ್ತಾವಿತ ವೆಚ್ಚಗಳನ್ನು ಮತ್ತು ಮಾಡಲಾದ ಬಟವಾಡೆಗಳ ವರದಿಯನ್ನು ಸೂಚಿಸಿ ಅದರ ಪ್ರತಿಯೊಂದು ಏಜೆನ್ಸಿಗೆ ಹಂಚಿಕೆ ಮಾಡಲಾದ ಆಯವ್ಯಯ.**

ಇದು ವಿಶೇಷ ಕಾರ್ಯದರ್ಶಿ(ಅಂರಾಜವಿ)ಯವರ ಆಪ್ತಶಾಖೆ ಆಗಿರುವುದರಿಂದ ಮೇಲೆ ಹೇಳಿರುವ ಕಾರ್ಯಗಳು ಸಂಬಂಧಪಡುವುದಿಲ್ಲ.

**4(1) ಬಿ (*xii*):– ಹಂಚಿಕೆ ಮಾಡಲಾದ ಮೊಬಲಗುಗಳನ್ನೊಳಗೊಂಡು, ಸಹಾಯ ಧನ ಕಾರ್ಯಕ್ರಮಗಳನ್ನು ಜಾರಿಯ ವಿಧಾನವನ್ನು ಮತ್ತು ಅಂತಹ ಕಾರ್ಯಕ್ರಮಗಳ ಫಲಾನುಭವಿಗಳ ವಿವರ:**

ಇದು ಆಪ್ತಶಾಖೆ ಆಗಿರುವುದರಿಂದ ಮೇಲೆ ಹೇಳಿರುವ ಕಾರ್ಯಗಳು ಸಂಬಂಧಪಡುವುದಿಲ್ಲ.

**4(1) ಬಿ (*xiii*):– ರಿಯಾಯಿತಿಗಳನ್ನು ಪಡೆಯುವವರ, ಅನುಮತಿಗಳು ಅಥವಾ ಸಾರ್ವಜನಿಕ ಪ್ರಾಧಿಕಾರದಿಂದ ಮಂಜೂರಾದ ಅಧಿಕಾರ ಪತ್ರಗಳ ವಿವರಗಳು:**

"ಅನ್ವಯಿಸುವುದಿಲ್ಲ"

**4(1) ಬಿ (*xiv*):– ವಿದ್ಯುನ್ಮಾನ ರೂಪದಲ್ಲಿ ಲಭ್ಯವಿರುವ ಇಲಾಖೆಯ ವಿವಿಧ ಯೋಜನೆಗಳ ವಿವರಗಳು ಮಾಹಿತಿಯನ್ನು ಒದಗಿಸುವುದು(ಫ್ಲಾಪಿ, ಸಿಡಿ, ವಿಸಿಡಿ, ವೆಬ್‌ಸೈಟ್ ಇಂಟರ್‌ನೆಟ್ ಇತ್ಯಾದಿ)**

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಗೆ ಸಂಬಂಧಪಟ್ಟ ಮಾಹಿತಿಗಳು ಇಲಾಖೆಯ ವೆಬ್‌ಸೈಟ್ www.karunadu.gov.in/law/home/aspx/ ನಲ್ಲಿ ಲಭ್ಯವಿರುತ್ತದೆ.

**4(1) ಬಿ (*xv*):– ಮಾಹಿತಿಯನ್ನು ಪಡೆಯಲು ನಾಗರೀಕರಿಗೆ ಲಭ್ಯವಿರುವ ಸೌಲಭ್ಯಗಳ ಬಗ್ಗೆ ವಿವರಗಳು.**

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಗೆ ಸಂಬಂಧಪಟ್ಟ ಮಾಹಿತಿಗಳು ಇಲಾಖೆಯ ವೆಬ್‌ಸೈಟ್ www.karunadu.gov.in/law/home/aspx/ ನಲ್ಲಿ ನಾಗರೀಕರು ಪಡೆದುಕೊಳ್ಳಬಹುದು. ಹಾಗೂ ಕರ್ನಾಟಕ ಮಾಹಿತಿ ಹಕ್ಕು ಕಾಯ್ದೆಯನ್ವಯ ಇಲಾಖೆಯ ವತಿಯಿಂದ ನೇಮಕಗೊಂಡ ಮಾಹಿತಿ ಅಧಿಕಾರಿಗಳ ಮೂಲಕ ಮಾಹಿತಿಗಳನ್ನು ಪಡೆದುಕೊಳ್ಳಬಹುದು.

**4(1) ಬಿ (*xvi*).– ಸಾರ್ವಜನಿಕರಿಗೆ ಮಾಹಿತಿ ಅಧಿಕಾರಿಗಳ ಹೆಸರುಗಳು, ಪದನಾಮಗಳು ಮತ್ತು ಇತರೆ ಮಾಹಿತಿ:**

| **ಸಾರ್ವಜನಿಕ ಮಾಹಿತಿ ಅಧಿಕಾರಿ ಮತ್ತು ವಿಳಾಸ** | **ಸಹಾಯಕ ಸಾರ್ವಜನಿಕ ಮಾಹಿತಿ ಅಧಿಕಾರಿ ಹೆಸರು ಮತ್ತು ವಿಳಾಸ** | **ಮೇಲ್ಮನವಿ ಪ್ರಾಧಿಕಾರಿಯ ಹೆಸರು ಮತ್ತು ವಿಳಾಸ** |
|---|---|---|
| ಶ್ರೀ ಪ್ರೇಮಚಂದ್ರ<br>ಸರ್ಕಾರದ ಉಪ ಕಾರ್ಯದರ್ಶಿ,<br>ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆ(ಅಂರಾಜವಿ), ಕೊ. ಸಂ:201, 2ನೇ ಮಹಡಿ, ವಿಕಾಸಸೌಧ<br>ಇ.ಮೇಲ್: mspremachandra 53@ gmail.com | ಶ್ರೀ ಮಹದೇವಯ್ಯ ಮಠಪತಿ<br>ಶಾಖಾಧಿಕಾರಿ ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆ (ಅಂರಾಜವಿ), ಕೊಠಡಿ ಸಂಖ್ಯೆ: 201, 2ನೇ ಮಹಡಿ, ವಿಕಾಸಸೌಧ, ಬೆಂ.<br>ಇ.ಮೇಲ್: mahadev math @rediffmail.com | ಶ್ರೀ ಕೆ.ಜಿ.ವಿ.ಮೂರ್ತಿ,<br>ಸರ್ಕಾರದ ವಿಶೇಷ ಕಾರ್ಯದರ್ಶಿ<br>ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆ,<br>ಕೊಠಡಿ ಸಂಖ್ಯೆ: 36, ನೆಲಮಹಡಿ, ವಿಧಾನಸೌಧ, ಬೆಂಗಳೂರು. |

**4(1) ಬಿ (*xvii*).– ವಿಶೇಷ ಕಾರ್ಯದರ್ಶಿ (ಅಂರಾಜವಿ) ನಿಯಮಿಸಬಹುದಾದಂತಹ ಇತರ ಮಾಹಿತಿ ಪ್ರಕಟಣೆಗೆ ಒಳಪಡುವಂತದ್ದು ಯಾವುದು ಇರುವುದಿಲ್ಲ.**

**4(1) ಬಿ (*i*).– ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯ ಅಪರ ಕಾನೂನು ಕಾರ್ಯದರ್ಶಿ (ಅಭಿಪ್ರಾಯ) ರವರ ಆಪ್ತ ಶಾಖೆಯ ರಚನೆ.**




**ಕಾರ್ಯಗಳು ಮತ್ತು ಕರ್ತವ್ಯಗಳು:**

ಸಚಿವಾಲಯದ ಇತರೆ ಇಲಾಖೆಗಳಿಂದ ಅಭಿಪ್ರಾಯ ಕೋರಿ ಬರುವ ಕಡತಗಳನ್ನು ಪರಿಶೀಲಿಸಿ ಅಭಿಪ್ರಾಯ ನೀಡುವುದು. ಮೇಲಾಧಿಕಾರಿಗಳು ಸೂಚಿಸಿದ ಕೆಲಸಗಳನ್ನು ನಿರ್ವಹಿಸುವುದು.

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯ ಅಭಿಪ್ರಾಯ ಶಾಖೆಗಳ ವಿಷಯಗಳಿಗೆ ಸಂಬಂಧಿಸಿದ ಅಪರ ಕಾರ್ಯದರ್ಶಿ(ಅಭಿಪ್ರಾಯ) ರವರ ಹುದ್ದೆಗೆ ಪೂರಕ ಸಿಬ್ಬಂದಿ ಈ ಆಪ್ತ ಶಾಖೆಯಲ್ಲಿ ಈ ಕೆಳಕಂಡಂತೆ ಕಾರ್ಯನಿರ್ವಹಿಸುತ್ತಾರೆ.

1. ಅಪರ ಕಾರ್ಯದರ್ಶಿ(ಅಭಿಪ್ರಾಯ), ರವರ ಆಪ್ತ ಶಾಖೆಯಿಂದ ಸ್ವೀಕರಿಸಲಾಗುವ ಪತ್ರಗಳು ಹಾಗೂ ಕಡತಗಳ ನಿರ್ವಹಣೆ.
2. ಅಧೀನಾಧಿಕಾರಿಯವರಿಂದ ಸ್ವೀಕೃತವಾಗುವ ಪ್ರಸ್ತಾವನೆಗಳನ್ನು ಅಪರ ಕಾರ್ಯದರ್ಶಿ (ಅಭಿಪ್ರಾಯ)ಯವರ ಪರಿಶೀಲನೆ ನಂತರ ಸಂಬಂಧಪಟ್ಟ ವಿಭಾಗಗಳಿಗೆ/ಶಾಖೆಗಳಿಗೆ ರವಾನಿಸುವುದು.
3. ಅಪರ ಕಾರ್ಯದರ್ಶಿ(ಅಭಿಪ್ರಾಯ)ರವರ ಉಕ್ತಲೇಖನವನ್ನು ಶೀಘ್ರಲಿಪಿಯಲ್ಲಿ ಬರೆದುಕೊಳ್ಳುವುದು ಹಾಗೂ ಅದನ್ನು ಸಂಬಂಧಪಟ್ಟ ಕಡತದಲ್ಲಿ ದಾಖಲಿಸಿ ನೀಡುವುದು.
4. ಅಧಿಕಾರಿಯ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ಮಾಹಿತಿ ನಿರ್ವಹಣೆ.
5. ಆಪ್ತ ಶಾಖೆಗೆ ಸಚಿವಾಲಯ ಕೈಪಿಡಿಯಲ್ಲಿ ವಹಿಸಿರುವ ಇತರೆ ಕಾರ್ಯಗಳು.

4(1)ಬಿ(*ii*) :- **ಅಧಿಕಾರಿ ಮತ್ತು ನೌಕರರುಗಳ ಹೊಣೆಗಾರಿಕೆ ಮತ್ತು ಕರ್ತವ್ಯಗಳು**

| | |
|---|---|
| 1) ಪತ್ರಾಂಕಿತ ಆಪ್ತ ಸಹಾಯಕರು : | ಸರ್ಕಾರದ ಅಪರ ಕಾರ್ಯದರ್ಶಿ(ಅಭಿಪ್ರಾಯ)ಯವರ ಆದೇಶದ ಮೇರೆಗೆ ಉಕ್ತಲೇಖನವನ್ನು ತೆಗದುಕೊಂಡು ಅದನ್ನು ಶೀಘ್ರವಾಗಿ ಗಣಕಯಂತ್ರದಲ್ಲಿ ಬೆರಳಚ್ಚಿಸಿ ಸಲ್ಲಿಸುವುದು. ದೂರವಾಣಿ ಕರೆಗಳನ್ನು ಸ್ವೀಕರಿಸಿ ವಿಶೇಷ ಕಾರ್ಯದರ್ಶಿಯವರಿಗೆ ಸಂಪರ್ಕ ಕಲ್ಪಿಸುವುದು. ಸಂದರ್ಶಕರು ಬಂದಾಗ ಭೇಟಿಗೆ ಏರ್ಪಾಡು ಮಾಡುವುದು. ಅಧಿಕಾರಿಗಳ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ನಿಖರವಾದ ಮಾಹಿತಿಗಳನ್ನು ಪಟ್ಟಿ ಮಾಡಿ ಅವುಗಳನ್ನು ಅನುಸರಿಸುವಂತೆ ಸಕಾಲದಲ್ಲಿ ಅಧಿಕಾರಿಯವರಿಗೆ ನೆನಪು ಮಾಡುವುದು. ಅಪರ ಕಾರ್ಯದರ್ಶಿ (ಅಭಿಪ್ರಾಯ) ಯವರಿಂದ ಸೂಚಿಸಲ್ಪಟ್ಟ ಇತರೆ ಕಛೇರಿ ಕೆಲಸಗಳು. ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಆಪ್ತ ಶಾಖೆಯ ಇನ್ನಿತರೆ ಕೆಲಸಗಳು.<br><br>ಅಪರ ಕಾರ್ಯದರ್ಶಿ(ಅಭಿಪ್ರಾಯ)ಯವರ ಅಧೀನದಲ್ಲಿ ಬರುವ ಕಾರ್ಯನಿರತ ವಿಭಾಗಗಳ ಉಪ ಕಾರ್ಯದರ್ಶಿ / ಶಾಖಾಧಿಕಾರಿಗಳಿಂದ ಸ್ವೀಕೃತವಾಗುವ ಕಡತಗಳನ್ನು ಅಪರ ಕಾರ್ಯದರ್ಶಿ (ಅಭಿಪ್ರಾಯ) ರವರಿಗೆ ಸಲ್ಲಿಸುವುದು. |
| 2) ಕಿರಿಯ ಸಹಾಯಕರು : | ಸರ್ಕಾರದ ಅಪರ ಕಾರ್ಯದರ್ಶಿ(ಅಭಿಪ್ರಾಯ)ಯವರಿಗೆ ವಿಳಾಸಿಸಿರುವ ಪತ್ರಗಳನ್ನು / ಕಡತಗಳನ್ನು ಸ್ವೀಕರಿಸಿದ ಕೂಡಲೇ ಸಹಾಯಕರ ವಹಿಯಲ್ಲಿ ನೋಂದಾಯಿಸುವುದು ನಂತರ ರವಾನಿಸುವುದು. ನಿಗದಿತ ತ:ಖ್ತೆಗಳ, ನಿಯತಕಾಲಿಕ ಸವಿವರಣೆಗಳ ತಯಾರಿಕೆ. ಅಧೀನ ಅಧಿಕಾರಿಗಳಿಂದ ಅಪರ ಕಾರ್ಯದರ್ಶಿಯವರಿಗೆ ಬರುವ ಕಡತ ಮತ್ತು ಪತ್ರಗಳನ್ನು ಗಣಕಯಂತ್ರ (ಎಲ್.ಎಂ.ಎಸ್. ಹಾಗೂ ಎಫ್.ಎಂ.ಎಸ್.) ಚಲನವಲನ ನಿರ್ವಹಣೆ. ಮೇಲಧಿಕಾರಿಗಳು ಸೂಚಿಸುವ ಇನ್ನಿತರೆ ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಇನ್ನಿತರೆ ಕೆಲಸಗಳು. |
| 3) ದಲಾಯತ್ : | ಕಛೇರಿಯನ್ನು ಅಚ್ಚುಕಟ್ಟಾಗಿ ಚೊಕ್ಕಟವಾಗಿಡುವುದು. ಅಪರ ಕಾರ್ಯದರ್ಶಿಯವರ ಕರೆಗಂಟೆಗೆ ಓಗೊಡುವುದು. ಇತರೆ ಶಾಖೆಗಳಿಗೆ /ಇಲಾಖೆಗಳಿಗೆ ಕಡತಗಳನ್ನು ಹಾಗೂ ಟಪಾಲುಗಳನ್ನು ಖುದ್ದಾಗಿ ತಲುಪಿಸುವುದು. ಕಛೇರಿಯ ಮೇಲಧಿಕಾರಿಗಳು ಸೂಚಿಸುವ ಕೆಲಸಗಳು ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಇನ್ನಿತರೆ ಕೆಲಸಗಳ ನಿರ್ವಹಣೆ. |
| 4) ವಾಹನ ಚಾಲಕರು : | ಅಪರ ಕಾರ್ಯದರ್ಶಿಯವರ ಕಛೇರಿ ಉಪಯೋಗಕ್ಕಿರುವ ಸರ್ಕಾರದ ಅಧಿಕೃತ ವಾಹನವನ್ನು ನಿರ್ವಹಿಸುವುದು ಹಾಗೂ ಚಾಲಿಸುವುದು. ವಾಹನದ ಲಾಗ್ ಪುಸ್ತಕ ನಿರ್ವಹಣೆ ಹಾಗೂ ವಾಹನವನ್ನು ಸುಸ್ಥಿತಿಯಲ್ಲಿಡುವುದು. ಸಚಿವಾಲಯದ ಕೈಪಿಡಿಯಲ್ಲಿ ಸೂಚಿಸಿರುವಂತೆ ಚಾಲಕರ ಕರ್ತವ್ಯಗಳನ್ನು ನಿರ್ವಹಿಸುವುದು. |

**4(1)ಬಿ(*iii*):– ಮೇಲ್ವಿಚಾರಣೆ ಮತ್ತು ಹೊಣೆಗಾರಿಕೆಯ ಮಾರ್ಗಗಳು ಸೇರಿದಂತೆ ತೀರ್ಮಾನ ತೆಗೆದುಕೊಳ್ಳುವ ಪ್ರಕ್ರಿಯೆಯಲ್ಲಿ ಅನುಸರಿಸಬೇಕಾದ ಕಾರ್ಯವಿಧಾನ:**

1. ಪತ್ರಾಂಕಿತ ಆಪ್ತ ಸಹಾಯಕರು:– ಅಪರ ಕಾರ್ಯದರ್ಶಿ (ಅಭಿಪ್ರಾಯ) ಯವರ ಆಪ್ತ ಸಹಾಯಕರಾಗಿ ಅವರ ಸಲಹೆ ಹಾಗೂ ಸೂಚನೆಯ ಮೇರೆಗೆ ಬೆರಳಚ್ಚು, ಕಾರ್ಯಕ್ರಮ ಪಟ್ಟಿ ಹಾಗೂ ದಿನಚರಿ ಒಳಗೊಂಡಂತೆ ಆಪ್ತ ಶಾಖೆಯ ಕಛೇರಿ ಕಾರ್ಯಗಳನ್ನು ನಿರ್ವಹಿಸುವುದು.

2. ಕಿರಿಯ ಸಹಾಯಕರು:– ಕರ್ನಾಟಕ ಸರ್ಕಾರ ಸಚಿವಾಲಯ ಕೈಪಿಡಿಯಲ್ಲಿ ಸೂಚಿಸಿರುವಂತೆ ಸರ್ಕಾರದ ಅಪರ ಕಾರ್ಯದರ್ಶಿಯವರಿಗೆ ಬರುವ ಎಲ್ಲಾ ಕಡತಗಳ ಮತ್ತು ಪತ್ರಗಳ ನಿರ್ವಹಣೆ ಹಾಗೂ ಚಲನವಲನ ನಮೂದನ್ನು ಸಂಬಂಧಿಸಿದ ವಹಿಗಳಲ್ಲಿ ನೋಂದಾಯಿಸಿ ಅವುಗಳ ರವಾನೆ ಕಾರ್ಯಗಳನ್ನು ಅಂದಂದೇ ನಿರ್ವಹಿಸುವುದು.

3. ದಲಾಯತ್:– ಕಛೇರಿಯ ಸಮಯಕ್ಕೆ ಮುಂಚೆಯೇ ಹಾಜರಾಗಿ ಕಛೇರಿಯನ್ನು ಸ್ವಚ್ಛವಾಗಿಡುವುದು. ಕಡತ / ಟಪಾಲುಗಳನ್ನು ಸಂಬಂಧಪಟ್ಟ ವಿಭಾಗ / ಶಾಖೆಗಳಿಗೆ ಕೂಡಲೇ ಅಂದಂದೇ ತಲುಪಿಸುವುದು.

**4(1)ಬಿ(*iv*):– ಕರ್ತವ್ಯ ನಿರ್ವಹಿಸುವಲ್ಲಿ ಅನುಸರಿಸಬೇಕಾದ ಮಾದರಿ/ ಗೊತ್ತುಪಡಿಸಿದ ನಿಗದಿಪಡಿಸಿರುವ ಮಾರ್ಗಸೂಚಿಗಳು:**

2005ರ ಕರ್ನಾಟಕ ಸರ್ಕಾರ ಸಚಿವಾಲಯದ ಪರಿಷ್ಕೃತ ಕೈಪಿಡಿ, ಸಚಿವಾಲಯ ವಾಹಿನಿ ಹಾಗೂ ಕರ್ನಾಟಕ ಸರ್ಕಾರದ(ವ್ಯವಹಾರ ಹಂಚಿಕೆ) ನಿಯಮಗಳು, 1977 ಹಾಗೂ ಕಾಲಕಾಲಕ್ಕೆ ಸಿಬ್ಬಂದಿ ಮತ್ತಿತರ ಆಡಳಿತ ಸುಧಾರಣೆ ಇಲಾಖೆಗಳಿಂದ ಹೊರಡಿಸಲಾಗುವ ಆದೇಶ, ಇತರೆ ಸರ್ಕಾರಿ ಆದೇಶಗಳು ಮತ್ತು ಸುತ್ತೋಲೆಗಳು. ಅಭಿಪ್ರಾಯಕ್ಕಾಗಿ ಆಡಳಿತ ಇಲಾಖೆಯಿಂದ ಸಲ್ಲಿಸುವ ಕಡತಗಳ ಪ್ರಕರಣಕ್ಕೆ ಸಂಬಂಧಿಸಿದ ಎಲ್ಲಾ ಕಾಯಿದೆ,

ನಿಯಮ ಮಾನ್ಯ ಸರ್ವೋಚ್ಚ ನ್ಯಾಯಾಲಯದ ತೀರ್ಪು, ಮಾನ್ಯ ಕರ್ನಾಟಕ ಉಚ್ಚ ನ್ಯಾಯಾಲಯದ ತೀರ್ಪು, ಭಾರತ ದೇಶದ ಬೇರೆ ರಾಜ್ಯಗಳ ಉಚ್ಚ ನ್ಯಾಯಾಲಯದ ತೀರ್ಪುಗಳು ಹಾಗೂ ಕಾನೂನಿನ ಅನ್ವಯ ಸ್ಥಾಪಿತವಾದ ಇತರ ನ್ಯಾಯಾಲಯಗಳ ತೀರ್ಪು ಇತ್ಯಾದಿ.

**4(1)ಬಿ(*v*) :– ಸಿಬ್ಬಂದಿ/ಅಧಿಕಾರಿಗಳು ಕರ್ತವ್ಯ ನಿರ್ವಹಣೆಯಲ್ಲಿ ಬಳಸುವ ನಿಯಮಗಳ, ಕಾಯಿದೆಗಳ ಮತ್ತು ಸೂಚನೆಗಳ ಕೈಪಿಡಿಗಳ ವಿವರ:**

1 2005 ಕರ್ನಾಟಕ ಸರ್ಕಾರ ಸಚಿವಾಲಯದ ಪರಿಷ್ಕೃತ ಕೈಪಿಡಿ
2 ಮಾಹಿತಿ ಹಕ್ಕು ಅಧಿನಿಯಮ 2005
3 ಕರ್ನಾಟಕ ನಾಗರೀಕ ಸೇವಾ ನಿಯಮಗಳು 1958
4 ಕರ್ನಾಟಕ ಸಾದಿಲ್ವಾರು ವೆಚ್ಚದ ಕೈಪಿಡಿ, 1958
5 ಕರ್ನಾಟಕ ಸರ್ಕಾರದ (ವ್ಯವಹಾರ ಹಂಚಿಕೆ) ನಿಯಮಗಳು 1977
6 ಕರ್ನಾಟಕ ಸಾರ್ವಜನಿಕ ಸಂಗ್ರಹಣೆಯಲ್ಲಿ ಪಾರದರ್ಶಕತೆ ಅಧಿನಿಯಮ – 1999
7 ಕರ್ನಾಟಕ ಸಾರ್ವಜನಿಕ ಸಂಗ್ರಹಣೆಯಲ್ಲಿ ಪಾರದರ್ಶಕತೆ (ತಿದ್ದುಪಡಿ) ಅಧಿನಿಯಮ – 2001
8 ಆರ್ಥಿಕ ಇಲಾಖೆಯಿಂದ ಕಾರ್ಯದರ್ಶಿಯವರಿಗೆ ಪ್ರತ್ಯಾಯೋಜಿಸಿರುವ ಆರ್ಥಿಕ ಅಧಿಕಾರದ ಆದೇಶಗಳು.
9 ಕರ್ನಾಟಕ ನ್ಯಾಯಾಂಗ ಅಧಿಕಾರಿಗಳ (ವೈದ್ಯಕೀಯ ಹಾಜರಾತಿ) ನಿಯಮಗಳು, 2009
10 ಕರ್ನಾಟಕ ಸರ್ಕಾರಿ ನೌಕರರ (ವೈದ್ಯಕೀಯ ಹಾಜರಾತಿ) ನಿಯಮಗಳು, 1963
11 ಕರ್ನಾಟಕ ನಾಗರೀಕ ಸೇವೆಗಳು (ಸಾಮಾನ್ಯ ನೇಮಕಾತಿ) ನಿಯಮಗಳು, 1977
12 ಕರ್ನಾಟಕ ನಾಗರೀಕ ಸೇವೆಗಳು (ನಡತೆ) ನಿಯಮಗಳು, 1966
13 ಕರ್ನಾಟಕ ನಾಗರೀಕ ಸೇವೆಗಳು (ಸಿ.ಸಿ.ಎ) ನಿಯಮಗಳು, 1957
14 ಕರ್ನಾಟಕ ಆರ್ಥಿಕ ಸಂಹಿತೆ, 1958
15 ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ ಹಾಗೂ ಆರ್ಥಿಕ ಇಲಾಖೆ ಹೊರಡಿಸಿರುವ ಆದೇಶ / ಸುತ್ತೋಲೆ
16 ಕರ್ನಾಟಕ ಕಾನೂನು ಅಧಿಕಾರಿಗಳ (ನೇಮಕಾತಿ ಮತ್ತು ಸೇವಾ ಷರತ್ತುಗಳು) ನಿಯಮಗಳು, 1977
17 ನೋಟರಿ ಅಧಿನಿಯಮ ಮತ್ತು ನಿಯಮಗಳು
18 ದಿ ಕರ್ನಾಟಕ ಕಂಡಕ್ಟ್ ಆಫ್ ಗೌರ್ನಮೆಂಟ್ ಲಿಟಿಗೇಷನ್ ರೂಲ್ಸ್, 1985

**4(1)ಬಿ(*vi*) :– ನಿಯಂತ್ರಣದಲ್ಲಿರುವ ದಸ್ತಾವೇಜುಗಳ ಪ್ರವರ್ಗಗಳ ವಿವರ ಪಟ್ಟಿ:**

ಸಚಿವಾಲಯ ವಾಹಿನಿ ಮೇರೆಗೆ ಸಂಬಂಧಪಟ್ಟ ಶಾಖೆಗಳಲ್ಲಿ ಎಲ್ಲಾ ಕಡತಗಳು ಹಾಗೂ ಹಿಂದೆ ಮುಕ್ತಾಯಗೊಂಡಂತಹ ಪ್ರಮುಖ ಕಡತಗಳು ಲಭ್ಯವಿರುತ್ತದೆ. ಆಪ್ತ ಶಾಖೆಯಲ್ಲಿ ಯಾವುದೇ ಕಡತಗಳನ್ನು ಸೃಜಿಸುವುದಿಲ್ಲ.

**4(1)ಬಿ(*vii*):– ಕಾರ್ಯನೀತಿ ರಚನೆ ಅಥವಾ ಅನುಷ್ಠಾನಕ್ಕೆ ಸಂಬಂಧಿಸಿದಂತೆ ಸಾರ್ವಜನಿಕರೊಡನೆ ಸಮಾಲೋಚಿಸಲು ಅಥವಾ ಅವರ ಪ್ರಾತಿನಿಧ್ಯವಿರುವಂತೆ ಮಾಡಲು ಇರುವ ಯಾವುದೇ ವ್ಯವಸ್ಥೆಯ ವಿವರ:**

ಆಪ್ತ ಶಾಖೆಯಲ್ಲಿ ಈ ತರಹದ ವ್ಯವಸ್ಥೆಯನ್ನು ಮಾಡಿಕೊಂಡಿರುವುದಿಲ್ಲ.

**4(1)ಬಿ(*viii*):– ಮಂಡಳಿಗಳು, ಪರಿಷತ್ತುಗಳು, ಸಮಿತಿಗಳು ಅಥವಾ ಅದರ ಭಾಗವಾಗಿ ಅಥವಾ ಅದರ ಸಲಹೆಯ ಉದ್ದೇಶಕ್ಕಾಗಿ ರಚಿತವಾದ ಇಬ್ಬರು ಅಥವಾ ಹೆಚ್ಚು ವ್ಯಕ್ತಿಗಳನ್ನೊಳಗೊಂಡ ಮಂಡಳಿಗಳ, ಪರಿಷತ್ತುಗಳ ಸಮಿತಿಗಳ ಮತ್ತು ಇತರ ನಿಕಾಯಗಳ ಸಭೆಗಳು ಸಾರ್ವಜನಿಕರಿಗೆ ಮುಕ್ತವಾಗಿರುತ್ತವೆಯೋ ಅಥವಾ ಅಂತಹ ಸಭೆಗಳ ನಡವಳಿಗಳು ಸಾರ್ವಜನಿಕರಿಗೆ ದೊರಕುತ್ತವೆಯೋ ಎಂಬುದರ ವಿವರ ಪಟ್ಟಿ:**

ಇದು ಆಪ್ತಶಾಖೆಯಾಗಿರುವುದರಿಂದ ಇಲ್ಲಿ ಮೇಲೆ ಹೇಳಿರುವ ವಿವರಗಳ ಪಟ್ಟಿ ಲಭ್ಯವಿರುವುದಿಲ್ಲ. ಸಾರ್ವಜನಿಕರು ಈ ತರಹದ ಮಾಹಿತಿಗಳನ್ನೇನಾದರೂ ಕೇಳಿದರೆ ಅವರಿಗೆ ಸಂಬಂಧಪಟ್ಟ ಶಾಖೆಗಳನ್ನು ಸಂಪರ್ಕಿಸಲು ತಿಳಿಸಲಾಗುವುದು.

**4(1) ಬಿ (*ix*) & (*x*):– ಅಪರ ಕಾರ್ಯದರ್ಶಿ (ಅಭಿಪ್ರಾಯ) ಹಾಗೂ ಆಪ್ತ ಶಾಖೆಯ ನೌಕರರ ಮಾಹಿತಿ ಹಾಗೂ ಪಡೆಯುತ್ತಿರುವ ವೇತನ.**

| ಕ್ರಮ ಸಂಖ್ಯೆ | ಹುದ್ದೆ | ಹೆಸರು ಶ್ರೀ/ಶ್ರೀಮತಿ | ದೂರವಾಣಿ ಸಂಖ್ಯೆ | ಮಾಸಿಕ ವೇತನ |
|---|---|---|---|---|
| 1. | ಸರ್ಕಾರದ ಅಪರ ಕಾರ್ಯದರ್ಶಿ (ಅಭಿಪ್ರಾಯ) | ಎಂ. ಶ್ರೀದೇವಿ | 22251996 | 95,546-00 |
| 2. | ಪತ್ರಾಂಕಿತ ಆಪ್ತ ಸಹಾಯಕರು | ಎಂ.ಕೆ. ಉಷಾ | 22251996 | 43,940-00 |
| 3. | ಕಿರಿಯ ಸಹಾಯಕರು | ಶಿವಪ್ಪ | 22251996 | 16,075-00 |
| 4. | ಜಮೇದಾರ್ | ದೊರೆಮಾಣಿಕ್ಯಂ | 22251996 | 21,550-00 |
| 5. | ವಾಹನ ಚಾಲಕರು | ಸಾದಿಕ್‌ವುಲ್ಲಾ | 22251996 | 13,385 |

**4(1) ಬಿ (*xi*):– ಎಲ್ಲಾ ಯೋಜನೆಗಳ ವಿವರಗಳನ್ನು ಸೂಚಿಸುವ ಪ್ರಸ್ತಾವಿತ ವೆಚ್ಚಗಳನ್ನು ಮತ್ತು ಮಾಡಲಾದ ಬಟವಾಡೆಗಳ ವರದಿಯನ್ನು ಸೂಚಿಸಿ ಅದರ ಪ್ರತಿಯೊಂದು ಏಜೆನ್ಸಿಗೆ ಹಂಚಿಕೆ ಮಾಡಲಾದ ಆಯವ್ಯಯ.**

ಇದು ಅಪರ ಕಾರ್ಯದರ್ಶಿ(ಅಭಿಪ್ರಾಯ)ಯವರ ಆಪ್ತಶಾಖೆ ಆಗಿರುವುದರಿಂದ ಮೇಲೆ ಹೇಳಿರುವ ಕಾರ್ಯಗಳು ಸಂಬಂಧಪಡುವುದಿಲ್ಲ.

**4(1) ಬಿ (*xii*):– ಹಂಚಿಕೆ ಮಾಡಲಾದ ಮೊಬಲಗನ್ನೊಳಗೊಂಡು, ಸಹಾಯ ಧನ ಕಾರ್ಯಕ್ರಮಗಳನ್ನು ಜಾರಿಯ ವಿಧಾನವನ್ನು ಮತ್ತು ಅಂತಹ ಕಾರ್ಯಕ್ರಮಗಳ ಫಲಾನುಭವಿಗಳ ವಿವರ:**

ಇದು ಆಪ್ತಶಾಖೆ ಆಗಿರುವುದರಿಂದ ಮೇಲೆ ಹೇಳಿರುವ ಕಾರ್ಯಗಳು ಸಂಬಂಧಪಡುವುದಿಲ್ಲ.

**4(1) ಬಿ (*xiii*):– ರಿಯಾಯಿತಿಗಳನ್ನು ಪಡೆಯುವವರ, ಅನುಮತಿಗಳು ಅಥವಾ ಸಾರ್ವಜನಿಕ ಪ್ರಾಧಿಕಾರದಿಂದ ಮಂಜೂರಾದ ಅಧಿಕಾರ ಪತ್ರಗಳ ವಿವರಗಳು:**

"ಅನ್ವಯಿಸುವುದಿಲ್ಲ"

**4(1) ಬಿ (*xiv*):– ವಿದ್ಯುನ್ಮಾನ ರೂಪದಲ್ಲಿ ಲಭ್ಯವಿರುವ ಇಲಾಖೆಯ ವಿವಿಧ ಯೋಜನೆಗಳ ವಿವರಗಳು ಮಾಹಿತಿಯನ್ನು ಒದಗಿಸುವುದು (ಫ್ಲಾಪಿ, ಸಿಡಿ, ವಿಸಿಡಿ, ವೆಬ್‌ಸೈಟ್ ಇಂಟರ್‌ನೆಟ್ ಇತ್ಯಾದಿ)**

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಗೆ ಸಂಬಂಧಪಟ್ಟ ಮಾಹಿತಿಗಳು ಇಲಾಖೆಯ ವೆಬ್‌ಸೈಟ್ www.karunadu.gov.in/law/home/aspx/ ನಲ್ಲಿ ಲಭ್ಯವಿರುತ್ತದೆ.

**4(1) ಬಿ (*xv*):– ಮಾಹಿತಿಯನ್ನು ಪಡೆಯಲು ನಾಗರೀಕರಿಗೆ ಲಭ್ಯವಿರುವ ಸೌಲಭ್ಯಗಳ ಬಗ್ಗೆ ವಿವರಗಳು**

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಗೆ ಸಂಬಂಧಪಟ್ಟ ಮಾಹಿತಿಗಳು ಇಲಾಖೆಯ ವೆಬ್‌ಸೈಟ್ www.karunadu.gov.in/law/home/aspx/ ನಲ್ಲಿ ನಾಗರೀಕರು ಪಡೆದುಕೊಳ್ಳಬಹುದು. ಹಾಗೂ ಕರ್ನಾಟಕ ಮಾಹಿತಿ ಹಕ್ಕು ಕಾಯ್ದೆಯನ್ವಯ ಇಲಾಖೆಯ ವತಿಯಿಂದ ನೇಮಕಗೊಂಡ ಮಾಹಿತಿ ಅಧಿಕಾರಿಗಳ ಮೂಲಕ ಮಾಹಿತಿಗಳನ್ನು ಪಡೆದುಕೊಳ್ಳಬಹುದು.

**4(1) ಬಿ (*xvi*):– ಸಾರ್ವಜನಿಕರಿಗೆ ಮಾಹಿತಿ ಅಧಿಕಾರಿಗಳ ಹೆಸರುಗಳು, ಪದನಾಮಗಳು ಮತ್ತು ಇತರೆ ಮಾಹಿತಿ:**

| ಸಾರ್ವಜನಿಕ ಮಾಹಿತಿ ಅಧಿಕಾರಿ | ಸಹಾಯಕ ಸಾರ್ವಜನಿಕ ಮಾಹಿತಿ ಅಧಿಕಾರಿ | ಮೇಲ್ಮನವಿ ಪ್ರಾಧಿಕಾರ |
|---|---|---|
| 1) ಶ್ರೀ ಮೊಹಮ್ಮದ್ ಇಸ್ಮಾಹಿಲ್ ಸರ್ಕಾರದ ಉಪ ಕಾರ್ಯದರ್ಶಿ (ಅಭಿಪ್ರಾಯ–1) | ಶ್ರೀ ಪಿ.ನರಸಿಂಹಮೂರ್ತಿ, ಶಾಖಾಧಿಕಾರಿ (ಅಭಿಪ್ರಾಯ) | ಶ್ರೀಮತಿ ಎಂ. ಶ್ರೀದೇವಿ, ಅಪರ ಕಾನೂನು ಕಾರ್ಯದರ್ಶಿ (ಅಭಿಪ್ರಾಯ) |
| 2) ಶ್ರೀ ಜಿ.ಎಸ್.ಪ್ರಶೀಲ ಕುಮಾರಿ ಸರ್ಕಾರದ ಉಪ ಕಾರ್ಯದರ್ಶಿ (ಅಭಿಪ್ರಾಯ–2)<br>3) ಶ್ರೀ ಎಂ.ಮಹದೇವಯ್ಯ, ಸರ್ಕಾರದ ಉಪ ಕಾರ್ಯದರ್ಶಿ (ಅಭಿಪ್ರಾಯ–3) | ಶ್ರೀ ಪಿ.ನರಸಿಂಹಮೂರ್ತಿ, ಶಾಖಾಧಿಕಾರಿ (ಅಭಿಪ್ರಾಯ) | ಶ್ರೀಮತಿ ಎಂ.ಶ್ರೀದೇವಿ, ಅಪರ ಕಾನೂನು ಕಾರ್ಯದರ್ಶಿ (ಅಭಿಪ್ರಾಯ) |

**4(1) ಬಿ (*xvii*):– ಸಾರ್ವಜನಿಕರು ಪಡೆಯಬಹುದಾದಂತ ಇತರೆ ಉಪಯೋಗಿತ ಮಾಹಿತಿಗಳು:**

ಅಪರ ಕಾರ್ಯದರ್ಶಿ (ಅಭಿಪ್ರಾಯ) ನಿಯಮಿಸಬಹುದಾದಂತಹ ಇತರ ಮಾಹಿತಿ ಪ್ರಕಟಣೆಗೆ ಒಳಪಡುವಂತದ್ದು ಇರುವುದಿಲ್ಲ.

**4(1) ಬಿ (*i*):– ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯ ಅಪರ ಕಾನೂನು ಕಾರ್ಯದರ್ಶಿ–1 ರವರ ಆಪ್ತ ಶಾಖೆಯ ರಚನೆ.**



**ಕಾರ್ಯಗಳು ಮತ್ತು ಕರ್ತವ್ಯಗಳು:**

ಅಪರ ಕಾನೂನು ಕಾರ್ಯದರ್ಶಿ–Iರವರು ಕಾನೂನು ಕೋಶದ ಮುಖ್ಯಸ್ಥರುಗಳ ಸಹಾಯದಿಂದ ಸರ್ವೋಚ್ಚ ನ್ಯಾಯಾಲಯ, ಕರ್ನಾಟಕ ಉಚ್ಚ ನ್ಯಾಯಾಲಯ, ಮತ್ತು ಕರ್ನಾಟಕ ಆಡಳಿತ ನ್ಯಾಯ ಮಂಡಳಿ, ಇಲ್ಲಿ ಕಾನೂನು ವ್ಯಾಜ್ಯಗಳಿಗೆ ಸಂಬಂಧಿಸಿದ ವಿಷಯಗಳ ನಿರ್ವಹಿಸುವ ಜವಾಬ್ದಾರಿ ಹೊಂದಿರುತ್ತಾರೆ.

ಕಾನೂನು, ನ್ಯಾಯ ಮತ್ತು ಮಾನವ ಹಕ್ಕುಗಳ ಇಲಾಖೆಯ ವ್ಯಾಜ್ಯ ಶಾಖೆಗಳ ವಿಷಯಗಳಿಗೆ ಸಂಬಂಧಿಸಿದ ಅಪರ ಕಾರ್ಯದರ್ಶಿ–Iರವರ ಹುದ್ದೆಗೆ ಪೂರಕ ಸಿಬ್ಬಂದಿ ಈ ಆಪ್ತ ಶಾಖೆಯಲ್ಲಿ ಈ ಕೆಳಕಂಡಂತೆ ಕಾರ್ಯನಿರ್ವಹಿಸುತ್ತಾರೆ.

1. ಅಪರ ಕಾರ್ಯದರ್ಶಿ–Iರವರ ಆಪ್ತ ಶಾಖೆಯಲ್ಲಿ ಸ್ವೀಕರಿಸಲಾಗುವ ಪತ್ರಗಳು ಹಾಗೂ ಕಡತಗಳ ನಿರ್ವಹಣೆ.
2. ಅಧೀನಾಧಿಕಾರಿಯವರಿಂದ ಸ್ವೀಕೃತವಾಗುವ ಪ್ರಸ್ತಾವನೆಗಳನ್ನು ಅಪರ ಕಾರ್ಯದರ್ಶಿ–Iರವರು ಪರಿಶೀಲಿಸಿದ ನಂತರ ಸಂಬಂಧಪಟ್ಟ ವಿಭಾಗಗಳಿಗೆ/ಶಾಖೆಗಳಿಗೆ ರವಾನಿಸುವುದು.
3. ಅಪರ ಕಾರ್ಯದರ್ಶಿ–Iರವರು ನೀಡಿದ ಉಕ್ತಲೇಖನವನ್ನು ಶೀಘ್ರಲಿಪಿಯಲ್ಲಿ ಬರೆದುಕೊಳ್ಳುವುದು ಹಾಗೂ ಅದನ್ನು ಸಂಬಂಧಪಟ್ಟ ಕಡತದಲ್ಲಿ ದಾಖಲಿಸಿ ನೀಡುವುದು.
4. ಅಧಿಕಾರಿಯ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ಮಾಹಿತಿ ನಿರ್ವಹಣೆ.
5. ಆಪ್ತ ಶಾಖೆಗೆ ಸಚಿವಾಲಯ ಕೈಪಿಡಿಯಲ್ಲಿ ವಹಿಸಿರುವ ಇತರೆ ಕಾರ್ಯಗಳು.

**4(1)ಬಿ(*ii*) :– ಅಧಿಕಾರಿ ಮತ್ತು ನೌಕರರುಗಳ ಹೊಣೆಗಾರಿಕೆ ಮತ್ತು ಕರ್ತವ್ಯಗಳು**

| | |
|---|---|
| 1) ಶೀಘ್ರಲಿಪಿಗಾರರು : | ಸರ್ಕಾರದ ಅಪರ ಕಾರ್ಯದರ್ಶಿ–Iರವರ ಆದೇಶದ ಮೇರೆಗೆ ಉಕ್ತಲೇಖನವನ್ನು ತೆಗದುಕೊಂಡು ಅದನ್ನು ಶೀಘ್ರವಾಗಿ ಗಣಕಯಂತ್ರದಲ್ಲಿ ಬೆರಳಚ್ಚಿಸಿ ಸಲ್ಲಿಸುವುದು. ದೂರವಾಣಿ ಕರೆಗಳನ್ನು ಸ್ವೀಕರಿಸಿ ವಿಶೇಷ ಕಾರ್ಯದರ್ಶಿಯವರಿಗೆ ಸಂಪರ್ಕ ಕಲ್ಪಿಸುವುದು. ಸಂದರ್ಶಕರು ಬಂದಾಗ ಭೇಟಿಗೆ ಏರ್ಪಾಡು ಮಾಡುವುದು. ಅಧಿಕಾರಿಗಳ ಕಾರ್ಯಕಲಾಪ, ಸಭೆ ಮುಂತಾದವುಗಳ ಬಗ್ಗೆ ನಿಖರವಾದ ಮಾಹಿತಿಗಳನ್ನು ಪಟ್ಟಿ ಮಾಡಿ ಅವುಗಳನ್ನು ಅನುಸರಿಸುವಂತೆ ಸಕಾಲದಲ್ಲಿ ಅಧಿಕಾರಿಯವರಿಗೆ ನೆನಪು ಮಾಡುವುದು. ಅಪರ ಕಾರ್ಯದರ್ಶಿ(ಅಭಿಪ್ರಾಯ)ಯವರಿಂದ ಸೂಚಿಸಲ್ಪಟ್ಟ ಇತರೆ ಕಛೇರಿ ಕೆಲಸಗಳು. ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಆಪ್ತ ಶಾಖೆಯ ಇನ್ನಿತರೆ ಕೆಲಸಗಳು.<br>ಅಪರ ಕಾರ್ಯದರ್ಶಿ–Iರವರ ಅಧೀನದಲ್ಲಿ ಬರುವ ಕಾರ್ಯನಿರತ ವಿಭಾಗಗಳ ಉಪ ಕಾರ್ಯದರ್ಶಿ / ಅಧೀನ ಕಾರ್ಯದರ್ಶಿಗಳಿಂದ ಸ್ವೀಕೃತವಾಗುವ ಕಡತಗಳನ್ನು ಅಪರ ಕಾರ್ಯದರ್ಶಿ–Iರವರಿಗೆ ಸಲ್ಲಿಸುವುದು. |
| 2) ಕಿರಿಯ ಸಹಾಯಕರು : | ಸರ್ಕಾರದ ಅಪರ ಕಾರ್ಯದರ್ಶಿ–Iರವರಿಗೆ ವಿಳಾಸಿಸಿರುವ ಹಾಗೂ ಪ್ರಧಾನ ಕಾರ್ಯದರ್ಶಿಯವರಿಂದ ಬಂದಂತಹ ಪತ್ರಗಳನ್ನು / ಕಡತಗಳನ್ನು ಸ್ವೀಕರಿಸಿದ ಕೂಡಲೇ ಸಹಾಯಕರ ವಹಿಯಲ್ಲಿ ನೋಂದಾಯಿಸುವುದು ನಂತರ ರವಾನಿಸುವುದು. ನಿಗದಿತ ತ:ಖ್ತೆಗಳ, ನಿಯತಕಾಲಿಕ ಸವಿವರಣೆಗಳ ತಯಾರಿಕೆ. ಅಧೀನ ಅಧಿಕಾರಿಗಳಿಂದ ಅಪರ ಕಾರ್ಯದರ್ಶಿಯವರಿಗೆ ಬರುವ ಕಡತ ಮತ್ತು ಪತ್ರಗಳನ್ನು ಗಣಕಯಂತ್ರ(ಎಲ್.ಎಂ.ಎಸ್. ಹಾಗೂ ಎಫ್.ಎಂ.ಎಸ್.) ಚಲನವಲನ ನಿರ್ವಹಣೆ. ಮೇಲಧಿಕಾರಿಗಳು ಸೂಚಿಸುವ ಇನ್ನಿತರೆ ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಇನ್ನಿತರೆ ಕೆಲಸಗಳು. |
| 3) ದಲಾಯತ್ : | ಕಛೇರಿಯನ್ನು ಅಚ್ಚುಕಟ್ಟಾಗಿ ಚೊಕ್ಕಟವಾಗಿಡುವುದು. ಅಪರ ಕಾರ್ಯದರ್ಶಿಯವರ ಕರೆಗಂಟೆಗೆ ಓಗೊಡುವುದು. ಇತರೆ ಶಾಖೆಗಳಿಗೆ /ಇಲಾಖೆಗಳಿಗೆ ಕಡತಗಳನ್ನು ಹಾಗೂ ಟಪಾಲುಗಳನ್ನು ಖುದ್ದಾಗಿ ತಲುಪಿಸುವುದು. ಕಛೇರಿಯ ಮೇಲಧಿಕಾರಿಗಳು ಸೂಚಿಸುವ ಕೆಲಸಗಳು ಹಾಗೂ ಸಚಿವಾಲಯದ ಕೈಪಿಡಿಯಲ್ಲಿ ಈ ಹುದ್ದೆಗೆ ಸೂಚಿಸಿರುವಂತೆ ಇನ್ನಿತರೆ ಕೆಲಸಗಳ ನಿರ್ವಹಣೆ. |
| 4) ವಾಹನ ಚಾಲಕರು : | ಅಪರ ಕಾರ್ಯದರ್ಶಿಯವರ ಕಛೇರಿ ಉಪಯೋಗಕ್ಕಿರುವ ಸರ್ಕಾರದ ಅಧಿಕೃತ ವಾಹನವನ್ನು ನಿರ್ವಹಿಸುವುದು ಹಾಗೂ ಚಾಲಿಸುವುದು. ವಾಹನದ ಲಾಗ್ ಪುಸ್ತಕ ನಿರ್ವಹಣೆ ಹಾಗೂ ವಾಹನವನ್ನು ಸುಸ್ಥಿತಿಯಲ್ಲಿಡುವುದು. ಸಚಿವಾಲಯದ ಕೈಪಿಡಿಯಲ್ಲಿ ಸೂಚಿಸಿರುವಂತೆ ಚಾಲಕರ ಕರ್ತವ್ಯಗಳನ್ನು ನಿರ್ವಹಿಸುವುದು. |

**4(1)ಬಿ(*iii*):– ಮೇಲ್ವಿಚಾರಣೆ ಮತ್ತು ಹೊಣೆಗಾರಿಕೆಯ ಮಾರ್ಗಗಳು ಸೇರಿದಂತೆ ತೀರ್ಮಾನ ತೆಗೆದುಕೊಳ್ಳುವ ಪ್ರಕ್ರಿಯೆಯಲ್ಲಿ ಅನುಸರಿಸಬೇಕಾದ ಕಾರ್ಯವಿಧಾನ:**

1. ಪತ್ರಾಂಕಿತ ಆಪ್ತ ಸಹಾಯಕರು:– ಅಪರ ಕಾನೂನು ಕಾರ್ಯದರ್ಶಿ–Iರವರ ಆಪ್ತ ಸಹಾಯಕರಾಗಿ ಅವರ ಸಲಹೆ ಹಾಗೂ ಸೂಚನೆಯ ಮೇರೆಗೆ ಬೆರಳಚ್ಚು, ಕಾರ್ಯಕ್ರಮ ಪಟ್ಟಿ ಹಾಗೂ ದಿನಚರಿ ಒಳಗೊಂಡಂತೆ ಆಪ್ತ ಶಾಖೆಯ ಕಛೇರಿ ಕಾರ್ಯಗಳನ್ನು ನಿರ್ವಹಿಸುವುದು.

2. ಕಿರಿಯ ಸಹಾಯಕರು:– ಕರ್ನಾಟಕ ಸರ್ಕಾರ ಸಚಿವಾಲಯ ಕೈಪಿಡಿಯಲ್ಲಿ ಸೂಚಿಸಿರುವಂತೆ ಸರ್ಕಾರದ ಅಪರ ಕಾನೂನು ಕಾರ್ಯದರ್ಶಿಯವರಿಗೆ ಬರುವ ಎಲ್ಲಾ ಕಡತಗಳ ಮತ್ತು ಪತ್ರಗಳ ನಿರ್ವಹಣೆ ಹಾಗೂ ಚಲನವಲನ ನಮೂದನ್ನು ಸಂಬಂಧಿಸಿದ ವಹಿಗಳಲ್ಲಿ ನೋಂದಾಯಿಸಿ ಅವುಗಳ ರವಾನೆ ಕಾರ್ಯಗಳನ್ನು ಅಂದಂದೇ ನಿರ್ವಹಿಸುವುದು.

3. ದಲಾಯತ್:– ಕಛೇರಿಯ ಸಮಯಕ್ಕೆ ಮುಂಚೆಯೇ ಹಾಜರಾಗಿ ಕಛೇರಿಯನ್ನು ಸ್ವಚ್ಛವಾಗಿಡುವುದು. ಕಡತ / ಟಪಾಲುಗಳನ್ನು ಸಂಬಂಧಪಟ್ಟ ವಿಭಾಗ / ಶಾಖೆಗಳಿಗೆ ಕೂಡಲೇ ಅಂದಂದೇ ತಲುಪಿಸುವುದು.

**4(1)ಬಿ(*iv*) :– ಕರ್ತವ್ಯ ನಿರ್ವಹಿಸುವಲ್ಲಿ ಅನುಸರಿಸಬೇಕಾದ ಮಾದರಿ/ ಗೊತ್ತುಪಡಿಸಿದ ನಿಗದಿಪಡಿಸಿರುವ ಮಾರ್ಗಸೂಚಿಗಳು:**

2005ರ ಕರ್ನಾಟಕ ಸರ್ಕಾರ ಸಚಿವಾಲಯದ ಪರಿಷ್ಕೃತ ಕೈಪಿಡಿ, ಸಚಿವಾಲಯ ವಾಹಿನಿ ಹಾಗೂ ಕರ್ನಾಟಕ ಸರ್ಕಾರದ(ವ್ಯವಹಾರ ಹಂಚಿಕೆ) ನಿಯಮಗಳು, 1977 ಹಾಗೂ ಕಾಲಕಾಲಕ್ಕೆ ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಗಳಿಂದ ಹೊರಡಿಸಲಾಗುವ ಆದೇಶ, ಇತರೆ ಸರ್ಕಾರಿ ಆದೇಶಗಳು ಮತ್ತು ಸುತ್ತೋಲೆಗಳು.

**4(1)ಬಿ(*v*) :– ಸಿಬ್ಬಂದಿ/ಅಧಿಕಾರಿಗಳು ಕರ್ತವ್ಯ ನಿರ್ವಹಣೆಯಲ್ಲಿ ಬಳಸುವ ನಿಯಮಗಳ, ಕಾಯಿದೆಗಳ ಮತ್ತು ಸೂಚನೆಗಳ ಕೈಪಿಡಿಗಳ ವಿವರ:**

1 2005 ಕರ್ನಾಟಕ ಸರ್ಕಾರ ಸಚಿವಾಲಯದ ಪರಿಷ್ಕೃತ ಕೈಪಿಡಿ
2 ಮಾಹಿತಿ ಹಕ್ಕು ಅಧಿನಿಯಮ 2005
3 ಕರ್ನಾಟಕ ನಾಗರೀಕ ಸೇವಾ ನಿಯಮಗಳು 1958
4 ಕರ್ನಾಟಕ ಸಾದಿಲ್ವಾರು ವೆಚ್ಚದ ಕೈಪಿಡಿ, 1958
5 ಕರ್ನಾಟಕ ಸರ್ಕಾರದ (ವ್ಯವಹಾರ ಹಂಚಿಕೆ) ನಿಯಮಗಳು 1977
6 ಕರ್ನಾಟಕ ಸಾರ್ವಜನಿಕ ಸಂಗ್ರಹಣೆಯಲ್ಲಿ ಪಾರದರ್ಶಕತೆ ಅಧಿನಿಯಮ – 1999
7 ಕರ್ನಾಟಕ ಸಾರ್ವಜನಿಕ ಸಂಗ್ರಹಣೆಯಲ್ಲಿ ಪಾರದರ್ಶಕತೆ (ತಿದ್ದುಪಡಿ) ಅಧಿನಿಯಮ – 2001
8 ಆರ್ಥಿಕ ಇಲಾಖೆಯಿಂದ ಕಾರ್ಯದರ್ಶಿಯವರಿಗೆ ಪ್ರತ್ಯಾಯೋಜಿಸಿರುವ ಆರ್ಥಿಕ ಅಧಿಕಾರದ ಆದೇಶಗಳು.
9 ಕರ್ನಾಟಕ ನ್ಯಾಯಾಂಗ ಅಧಿಕಾರಿಗಳ (ವೈದ್ಯಕೀಯ ಹಾಜರಾತಿ) ನಿಯಮಗಳು 2009
10 ಕರ್ನಾಟಕ ಸರ್ಕಾರಿ ನೌಕರರ (ವೈದ್ಯಕೀಯ ಹಾಜರಾತಿ) ನಿಯಮಗಳು, 1963
11 ಕರ್ನಾಟಕ ನಾಗರೀಕ ಸೇವೆಗಳು (ಸಾಮಾನ್ಯ ನೇಮಕಾತಿ) ನಿಯಮಗಳು, 1977
12 ಕರ್ನಾಟಕ ನಾಗರೀಕ ಸೇವೆಗಳು (ನಡತೆ) ನಿಯಮಗಳು, 1966
13 ಕರ್ನಾಟಕ ನಾಗರೀಕ ಸೇವೆಗಳು (ಸಿ.ಸಿ.ಎ) ನಿಯಮಗಳು, 1957
14 ಕರ್ನಾಟಕ ಆರ್ಥಿಕ ಸಂಹಿತೆ, 1958
15 ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ ಹಾಗೂ ಆರ್ಥಿಕ ಇಲಾಖೆ ಹೊರಡಿಸಿರುವ ಆದೇಶ / ಸುತ್ತೋಲೆ
16 ಕರ್ನಾಟಕ ಕಾನೂನು ಅಧಿಕಾರಿಗಳ (ನೇಮಕಾತಿ ಮತ್ತು ಸೇವಾ ಷರತ್ತುಗಳು) ನಿಯಮಗಳು, 1977
17 ನೋಟರಿ ಅಧಿನಿಯಮ ಮತ್ತು ನಿಯಮಗಳು
18 ದಿ ಕರ್ನಾಟಕ ಕಂಡಕ್ಟ್ ಆಫ್ ಗೌರ್ನಮೆಂಟ್ ಲಿಟಿಗೇಷನ್ ರೂಲ್ಸ್, 1985

**4(1)ಬಿ(*vi*):– ನಿಯಂತ್ರಣದಲ್ಲಿರುವ ದಸ್ತಾವೇಜುಗಳ ಪ್ರವರ್ಗಗಳ ವಿವರ ಪಟ್ಟಿ:**

ಸಚಿವಾಲಯ ವಾಹಿನಿ ಮೇರೆಗೆ ಸಂಬಂಧಪಟ್ಟ ಶಾಖೆಗಳಲ್ಲಿ ಎಲ್ಲಾ ಕಡತಗಳು ಹಾಗೂ ಹಿಂದೆ ಮುಕ್ತಾಯಗೊಂಡಂತಹ ಪ್ರಮುಖ ಕಡತಗಳು ಲಭ್ಯವಿರುತ್ತದೆ. ಆಪ್ತ ಶಾಖೆಯಲ್ಲಿ ಯಾವುದೇ ಕಡತಗಳನ್ನು ಸೃಜಿಸುವುದಿಲ್ಲ.

**4(1)ಬಿ(*vii*):– ಕಾರ್ಯನೀತಿ ರಚನೆ ಅಥವಾ ಅನುಷ್ಠಾನಕ್ಕೆ ಸಂಬಂಧಿಸಿದಂತೆ ಸಾರ್ವಜನಿಕರೊಡನೆ ಸಮಾಲೋಚಿಸಲು ಅಥವಾ ಅವರ ಪ್ರಾತಿನಿಧ್ಯವಿರುವಂತೆ ಮಾಡಲು ಇರುವ ಯಾವುದೇ ವ್ಯವಸ್ಥೆಯ ವಿವರ:**

ಆಪ್ತ ಶಾಖೆಯಲ್ಲಿ ಈ ತರಹದ ವ್ಯವಸ್ಥೆಯನ್ನು ಮಾಡಿಕೊಂಡಿರುವುದಿಲ್ಲ.

**4(1)ಬಿ(*viii*):– ಮಂಡಳಿಗಳು, ಪರಿಷತ್ತುಗಳು, ಸಮಿತಿಗಳು ಅಥವಾ ಅದರ ಭಾಗವಾಗಿ ಅಥವಾ ಅದರ ಸಲಹೆಯ ಉದ್ದೇಶಕ್ಕಾಗಿ ರಚಿತವಾದ ಇಬ್ಬರು ಅಥವಾ ಹೆಚ್ಚು ವ್ಯಕ್ತಿಗಳನ್ನೊಳಗೊಂಡ ಮಂಡಳಿಗಳ, ಪರಿಷತ್ತುಗಳ ಸಮಿತಿಗಳ ಮತ್ತು ಇತರ ನಿಕಾಯಗಳ ಸಭೆಗಳು ಸಾರ್ವಜನಿಕರಿಗೆ ಮುಕ್ತವಾಗಿರುತ್ತವೆಯೋ ಅಥವಾ ಅಂತಹ ಸಭೆಗಳ ನಡವಳಿಗಳು ಸಾರ್ವಜನಿಕರಿಗೆ ದೊರಕುತ್ತವೆಯೋ ಎಂಬುದರ ವಿವರ ಪಟ್ಟಿ:**

ಇದು ಆಪ್ತಶಾಖೆಯಾಗಿರುವುದರಿಂದ ಇಲ್ಲಿ ಮೇಲೆ ಹೇಳಿರುವ ವಿವರಗಳ ಪಟ್ಟಿ ಲಭ್ಯವಿರುವುದಿಲ್ಲ. ಸಾರ್ವಜನಿಕರು ಈ ತರಹದ ಮಾಹಿತಿಗಳನ್ನೇನಾದರೂ ಕೇಳಿದರೆ ಅವರಿಗೆ ಸಂಬಂಧಪಟ್ಟ ಶಾಖೆಗಳನ್ನು ಸಂಪರ್ಕಿಸಲು ತಿಳಿಸಲಾಗುವುದು.

